KA / BG-GPO / 2515 / WPP-47 / 2009-2011

# ಕರ್ನಾಟಕ ರಾಜ್ಯಪತ್ರ

**ಅಧಿಕೃತವಾಗಿ ಪ್ರಕಟಿಸಲಾದುದು**

| ಸಂಪುಟ ೧೪೪ | ಬೆಂಗಳೂರು, ಗುರುವಾರ, ಜುಲೈ ೧೬, ೨೦೦೯ (ಆಷಾಢ ೨೫, ಶಕ ವರ್ಷ ೧೯೩೧) | ಸಂಚಿಕೆ ೨೯ |
|---|---|---|

## ಭಾಗ – ೧

## ರಾಜ್ಯ ಸರ್ಕಾರದ ಮುಖ್ಯ ಆದೇಶಗಳು ಹಾಗೂ ಸುತ್ತೋಲೆ ಮುಂತಾದ ಎಲ್ಲಾ ಇಲಾಖೆಗಳಿಗೂ ಸಂಬಂಧಿಸಿದ ಆದೇಶಗಳು

### ಕನ್ನಡ ಮತ್ತು ಸಂಸ್ಕೃತಿ, ವಾರ್ತಾ ಮತ್ತು ಪ್ರವಾಸೋದ್ಯಮ ಸಚಿವಾಲಯ

**ವಿಷಯ:** ಶ್ರೀ ಎಂ.ಎಸ್. ಚಂದ್ರಪ್ಪ, ಸಹಾಯಕ ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಹಾಸನ ಇವರು ಲಂಚವನ್ನು ಸ್ವೀಕರಿಸುತಿದ್ದಾಗ ಲೋಕಾಯುಕ್ತಕ್ಕೆ ಸಿಕ್ಕಿಬಿದ್ದ ಕಾರಣ ಅಮಾನತಿನಲ್ಲಿಡುವ ಬಗ್ಗೆ

**ಓದಲಾಗಿದೆ:**
1. ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಇವರ ಪತ್ರ ಸಂಖ್ಯೆ: ಕಸನಿ:62:ಸಿಬ್ಬಂದಿ: 2008–09
2. ಅಪರ ಪೊಲೀಸ್ ಮಹಾ ನಿರ್ದೇಶಕರು, ಕರ್ನಾಟಕ ಲೋಕಾಯುಕ್ತ ಬೆಂಗಳೂರು ಅವರ ಪತ್ರ ಸಂಖ್ಯೆ: ಲೋಕ್/ಐಎನ್ವಿ(ಜಿ)/ಎಂ–11/ಸಿಆರ್–7/2009 ಹಾಸನ ದಿನಾಂಕ 13.03.2009

**ಪ್ರಸ್ತಾವನೆ:**

ಮೇಲೆ ಓದಲಾದ (1) ರ ಪತ್ರದಲ್ಲಿ ಶ್ರೀ ಎಂ.ಎಸ್. ಚಂದ್ರಪ್ಪ, ಸಹಾಯಕ ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಹಾಸನ ಜಿಲ್ಲೆಯ ಆಲೂರು ತಾಲ್ಲೂಕು, ಪಾಳ್ಯ ಹೋಬಳಿ ಕಾರ್ಜುಹಳ್ಳಿ ಗ್ರಾಮದ ವಾಸಿ ಶ್ರೀ ಕೆ.ಎನ್. ರಘು ಬಿನ್ ಎಸ್ ನಾಗರಾಜು ಅವರು ಶ್ರೀ ಮಂಜುನಾಥ ತೊಗಲು ಗೊಂಬೆ ಕಲಾಸಂಘದ ಕಾರ್ಯದರ್ಶಿಯಾಗಿದ್ದು, ತಮ್ಮ ಸಂಘದ ವತಿಯಿಂದ ಕನ್ನಡ ಮತ್ತು ಸಂಸ್ಕೃತಿ ಇಲಾಖೆಯ ಆಶ್ರಯದಲ್ಲಿ ದಿನಾಂಕ 19.02.2009ರಂದು ಆಲೂರು ತಾಲ್ಲೂಕು ಕಾರ್ಜುಹಳ್ಳಿ ಗ್ರಾಮದಲ್ಲಿ ತೊಗಲುಗೊಂಬೆ ಪ್ರದರ್ಶನವನ್ನು ನಡೆಸಿ ಕೊಟ್ಟಿದ್ದು, ಇದಕ್ಕಾಗಿ ಸರ್ಕಾರ ನೀಡುವ ರೂ. 10,000/– ಗಳ ಸಹಾಯ ಧನದ ಚೆಕ್ಕು ಕೊಡಲು ಶ್ರೀ ಎಂ.ಎಸ್, ಚಂದ್ರಪ್ಪ, ಸಹಾಯಕ ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಹಾಸನ ಇವರು ಸದರಿ ಫಿರ್ಯಾದು ಕಲಾವಿದರಿಂದ ರೂ.2,000/–ಗಳಿಗೆ ಒತ್ತಾಯಿಸಿ ರೂ.1,000/–ಲಂಚದ ಹಣವನ್ನು ದಿನಾಂಕ 03.03.2009ರಂದು ಸ್ವೀಕರಿಸುತ್ತಿದ್ದಾಗ ಲಂಚದ ಹಣದ ಸಮೇತ ಲೋಕಾಯುಕ್ತ ಪೊಲೀಸ್‌ರವರು ಬಂಧಿಸಿ ತನಿಖಾ ಕ್ರಮಗಳನ್ನು ಅನುಸರಿಸಿ ಗೌರವಾನ್ವಿತ ನ್ಯಾಯಾಲಯದಲ್ಲಿ ಹಾಜರು ಪಡಿಸಿರುತ್ತಾರೆ. ಹಾಗೂ ನ್ಯಾಯಾಲಯವು ದಿನಾಂಕ 04.03.2009ರವರೆಗೆ ನ್ಯಾಯಾಂಗ ಬಂಧನದಲ್ಲಿರಿಸಲು ಆದೇಶಿಸಿತ್ತು. ಈ ರೀತಿ ಶ್ರೀ ಎಂ.ಎಸ್. ಚಂದ್ರಪ್ಪ, ಸಹಾಯಕ ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಹಾಸನ ಇವರು ಕಲಾವಿದರಿಂದ ರೂ. 1,000/– ಲಂಚ ಸ್ವೀಕರಿಸಿದ್ದಕ್ಕಾಗಿ ಇವರ ಮೇಲೆ ಶಿಸ್ತಿನ ಕ್ರಮ ತೆಗೆದುಕೊಳ್ಳಲು ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆರವರು ಶಿಫಾರಸ್ಸು ಮಾಡಿರುತ್ತಾರೆ.

ಮೇಲೆ (2)ರಲ್ಲಿ ಓದಲಾದ ದಿನಾಂಕ 13.03.2009ರ ಪತ್ರದಲ್ಲಿ ಅಪರ ಪೊಲೀಸ್ ಮಹಾ ನಿರ್ದೇಶಕರು, ಕರ್ನಾಟಕ ಲೋಕಾಯುಕ್ತ ಬೆಂಗಳೂರು, ಇವರು ದಿನಾಂಕ 03.03.2009ರಂದು ಶ್ರೀ ಕೆ.ಎನ್. ರಘು ಬಿನ್ ಎಸ್ ನಾಗರಾಜು ಕಾರ್ಜುಹಳ್ಳಿ ಗ್ರಾಮ, ಪಾಳ್ಯ ಹೋಬಳಿ, ಆಲೂರು ತಾಲ್ಲೂಕು, ಹಾಸನ ಜಿಲ್ಲೆರವರು ಹಾಸನ ಲೋಕಾಯುಕ್ತ ಠಾಣೆಗೆ ಹಾಜರಾಗಿ ನೀಡಿದ ದೂರಿನ ಸಾರಾಂಶವೇನೆಂದರೆ ಫಿರ್ಯಾದುದಾರರು ಶ್ರೀ ಮಂಜುನಾಥ, ತೊಗಲು ಗೊಂಬೆ ಕಲಾಸಂಘದ ಕಾರ್ಯದರ್ಶಿಯಾಗಿದ್ದು, ತಮ್ಮ ಸಂಘದ ವತಿಯಿಂದ ಕನ್ನಡ ಮತ್ತು ಸಂಸ್ಕೃತಿ ಇಲಾಖೆಯ ಆಶ್ರಯದಲ್ಲಿ ದಿನಾಂಕ 19.02.2009ರಂದು ಆಲೂರು ತಾಲ್ಲೂಕು ಕಾರ್ಜುಹಳ್ಳಿ ಗ್ರಾಮದಲ್ಲಿ ತೊಗಲುಗೊಂಬೆ ಪ್ರದರ್ಶನವನ್ನು ನಡೆಸಿ

ಕೊಟ್ಟಿದ್ದು, ಇದಕ್ಕಾಗಿ ಸರ್ಕಾರ ನೀಡುವ ರೂ. 10,000/–ಗಳ ಸಹಾಯ ಧನದ ಚೆಕ್ಕು ಕೊಡಲು ಶ್ರೀ ಎಂ.ಎಸ್, ಚಂದ್ರಪ್ಪ, ಸಹಾಯಕ ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಹಾಸನ ಇವರು ಸದರಿ ಫಿರ್ಯಾದು ಕಲಾವಿದರಿಂದ ರೂ.2,000/–ಗಳಿಗೆ ಲಂಚದ ಹಣಕ್ಕಾಗಿ ಒತ್ತಾಯಿಸಿದ್ದು ಫಿರ್ಯಾದುದಾರರು ಅಷ್ಟು ಹಣ ಕೊಡಲು ಸಾಧ್ಯವಿಲ್ಲವೆಂದು ಹೇಳಿದಾಗ ಅವರು ಈಗ ರೂ.1,000/–ಕೊಡು, ಉಳಿದ ರೂ.1,000/–ಗಳನ್ನು ಬ್ಯಾಂಕಿನಲ್ಲಿ ಚೆಕ್ ಮೂಲಕ ಕ್ಯಾಷ್ ಮಾಡಿಕೊಂಡ ನಂತರ ತಂದು ಕೊಡುವಂತೆ ಒತ್ತಾಯಿಸಿರುತ್ತಾರೆ. ಫಿರ್ಯಾದುದಾರರಿಗೆ ಲಂಚ ಕೊಡಲು ಇಷ್ಟವಿಲ್ಲದ ಕಾರಣ ಸೂಕ್ತ ಕಾನೂನು ಕ್ರಮ ತೆಗೆದುಕೊಳ್ಳುವಂತೆ ಕೋರಿರುತ್ತಾರೆ. ಸದರಿ ದೂರಿನನ್ವಯ ಪೊಲೀಸ್ ನಿರೀಕ್ಷಕರು, ಕರ್ನಾಟಕ ಲೋಕಾಯುಕ್ತ ಪೊಲೀಸ್ ಠಾಣೆ, ಹಾಸನ ರವರು ಮೇಲ್ಕಂಡ ಅಧಿಕಾರಿಯವರ ವಿರುದ್ಧ ಭ್ರಷ್ಟಾಚಾರ ನಿರೋಧಕ ಕಾಯ್ದೆ 1988ರ ಕಲಂ 7,13(1)(ಡಿ) ಕೂಡ 13(2)ರ ಪ್ರಕಾರ ಹಾಸನ ಲೋಕಾಯುಕ್ತ ಠಾಣೆ ಮೊ.ನಂ. 07/2009 ರಲ್ಲಿ ಪ್ರಕರಣವನ್ನು ದಾಖಲು ಮಾಡಿಕೊಂಡು ದಿನಾಂಕ 03.03.2009ರಂದು ಬೀಸಿದ ಬಲೆಯು ಯಶಸ್ವಿಯಾಗಿದ್ದು, ಸದರಿ ಆರೋಪಿತ ಸರ್ಕಾರಿ ಅಧಿಕಾರಿಯವರಾದ ಶ್ರೀ ಎಂ.ಎಸ್.ಚಂದ್ರಪ್ಪ, ಸಹಾಯಕ ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಹಾಸನ ಇವರು ಫಿರ್ಯಾದುದಾರರಿಂದ ಲಂಚದ ಹಣ ರೂ.1,000/–ಗಳನ್ನು ಒತ್ತಾಯಿಸಿ ಸ್ವೀಕರಿಸಿ ಹಾಸನ ಲೋಕಾಯುಕ್ತ ಬಲೆಗೆ ಸಿಕಿಬಿದ್ದಿರುತ್ತಾರೆ. ಆರೋಪಿತರಿಂದ ಲಂಚದ ಹಣವನ್ನು ವಶಪಡಿಸಿಕೊಳ್ಳಲಾಗಿದೆಯೆಂದು ಹಾಗೂ ಆರೋಪಿತರನ್ನು ತನಿಖೆಯ ಸಲುವಾಗಿ ದಸ್ತಗಿರಿ ಮಾಡಲಾಗಿದೆ ಎಂದು ತಿಳಿಸಿರುತ್ತಾರೆ.

ಅಪರ ಮಹಾನಿರ್ದೇಶಕರು, ಕರ್ನಾಟಕ ಲೋಕಾಯುಕ್ತ, ಬೆಂಗಳೂರು ರವರು ಮೇಲೆ (2)ರ ತಮ್ಮ ಪತ್ರದಲ್ಲಿ ಸರ್ಕಾರದ ತಿದ್ದುಪಡಿ ಆದೇಶ ಸಂಖ್ಯೆ ಡಿಪಿಎಆರ್ 4 ಎಸ್.ಡಿ.ಇ 2000 ದಿನಾಂಕ 15.04.2002ನ್ನು ಉಲ್ಲೇಖಿಸುತ್ತಾ, ಶ್ರೀ ಎಂ.ಎಸ್.ಚಂದ್ರಪ್ಪ, ಸಹಾಯಕ ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಕಲಾಭವನ, ಹಾಸನ ರವರ ಮೇಲಿನ ಪ್ರಕರಣದ ಸುಗಮ ತನಿಖೆಗೆ ಅಡ್ಡಿ ಉಂಟು ಮಾಡುವ ಅಥವಾ ತನಿಖೆಯಲ್ಲಿ ಹಸ್ತಕ್ಷೇಪ ಮಾಡುವ ಹಾಗೂ ಸಾಕ್ಷಿ ಪುರಾವೆಗಳನ್ನು ನಾಶಗೊಳಿಸುವ ಸಾಧ್ಯತೆಗಳಿರುವುದರಿಂದ ಇವರನ್ನು ಈ ಕೂಡಲೇ ಅಮಾನತ್ತಿನಲ್ಲಿಡಬೇಕೆಂದು ಕೋರಿರುತ್ತಾರೆ. ಅಲ್ಲದೆ ಕೂಡಲೇ ಅವರ ಲೀನ್ (ಸ್ಥಾನ) ಅನ್ನು ಬೇರೆ ಕಡೆಗೆ ವರ್ಗಾಯಿಸಲು ಕೋರಿರುತ್ತಾರೆ.

ಮೇಲಿನ ಅಂಶಗಳ ಹಿನ್ನೆಲೆಯಲ್ಲಿ ಶ್ರೀ ಎಂ.ಎಸ್, ಚಂದ್ರಪ್ಪ, ಸಹಾಯಕ ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಹಾಸನ ಇವರನ್ನು ತಕ್ಷಣದಿಂದ ಜಾರಿಗೆ ಬರುವಂತೆ ಅಮಾನತ್ತಿನಲ್ಲಿಡಲು ಈ ಕೆಳಕಂಡ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಕಸಂವಾಪ್ರ 27 ಕಸನಿ 2009, ಬೆಂಗಳೂರು, ದಿನಾಂಕ: 18ನೇ ಮೇ 2009**

ಪ್ರಸ್ತಾವನೆಯಲ್ಲಿ ತಿಳಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಶ್ರೀ ಎಂ.ಎಸ್, ಚಂದ್ರಪ್ಪ, ಸಹಾಯಕ ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಹಾಸನ ಇವರ ವಿರುದ್ಧ ಪೊಲೀಸ್ ಇನ್ಸ್‌ಪೆಕ್ಟರ್, ಕರ್ನಾಟಕ ಲೋಕಾಯುಕ್ತ ಪೊಲೀಸ್ ಠಾಣೆ, ಹಾಸನ ರವರು ಭ್ರಷ್ಟಾಚಾರ ನಿರೋಧಕ ಕಾಯ್ದೆ 1988ರ ಕಲಂ 7,13(1)(ಡಿ) ಕೂಡ 13(2)ರ ಪ್ರಕಾರ ಹಾಸನ ಲೋಕಾಯುಕ್ತ ಪೊಲೀಸ್ ಠಾಣೆ ಮೊ.ನಂ. 07/2009 ರಲ್ಲಿ ಪ್ರಕರಣವನ್ನು ದಾಖಲು ಮಾಡಿದ್ದು ದಿನಾಂಕ 03.03.2009ರಂದು ರೂ.1,000/–ಗಳನ್ನು ಲಂಚವಾಗಿ ಸ್ವೀಕರಿಸುತ್ತಿದ್ದ ಸಂದರ್ಭದಲ್ಲಿ ಲೋಕಾಯುಕ್ತ ತನಿಖಾ ಅಧಿಕಾರಿಗಳು ಟ್ರ್ಯಾಪ್ ಮಾಡಿರುವುದರಿಂದ ಇವರ ವಿರುದ್ಧ ಹೂಡಲಾಗುವ ಇಲಾಖಾ ವಿಚಾರಣೆಯನ್ನು ಬಾಕಿ ಇಟ್ಟು, ಕರ್ನಾಟಕ ನಾಗರೀಕ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಮಗಳು 1957ರ ನಿಯಮ 10(1)(ಎ)ರ ಜೊತೆಯಲ್ಲಿ ಓದಲಾದ ಕರ್ನಾಟಕ ನಾಗರೀಕ ಸೇವಾ (ನಡತೆ) ನಿಯಮಗಳು 1966ರ ನಿಯಮ 3(1)(iii)ರ ಪ್ರಕಾರ ತಕ್ಷಣದಿಂದ ಜಾರಿಗೆ ಬರುವಂತೆ ಹಾಗೂ ಮುಂದಿನ ಆದೇಶದವರೆಗೆ ಸೇವೆಯಿಂದ ಅಮಾನತ್ತುಗೊಳಿಸಿದೆ.

ಶ್ರೀ ಎಂ.ಎಸ್, ಚಂದ್ರಪ್ಪ, ಸಹಾಯಕ ನಿರ್ದೇಶಕರು, ಕನ್ನಡ ಮತ್ತು ಸಂಸ್ಕೃತಿ ಇಲಾಖೆ, ಹಾಸನ ಇವರು ನಿಯಮಾನುಸಾರ ಜೀವನಾಧರ ಭತ್ಯೆ ಪಡೆಯಲು ಅರ್ಹರಿರುತ್ತಾರೆ. ಅಲ್ಲದೇ ಕೇಂದ್ರ ಸ್ಥಾನವನ್ನು ಪೂರ್ವಾನುಮತಿಯಿಲ್ಲದೆ ಬಿಡುವಂತಿಲ್ಲ ಎಂದು ಸರ್ಕಾರವು ಈ ಮೂಲಕ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಎಂ.ಕೆ.ಧರ್ಮರಾಜಪ್ಪ**

ಪಿ.ಆರ್. 1309

ಸರ್ಕಾರದ ಅಧೀನ ಕಾರ್ಯದರ್ಶಿ,

ಕನ್ನಡ ಮತ್ತು ಸಂಸ್ಕೃತಿ, ವಾರ್ತಾ ಮತ್ತು ಪ್ರವಾಸೋದ್ಯಮ ಇಲಾಖೆ (ಆಡಳಿತ ಕನ್ನಡ).

**ವಿಷಯ:** ಸ್ವತಂತ್ರ ಮೌಲ್ಯಮಾಪನ ಪ್ರಕ್ರಿಯೆಗಾಗಿ ಇಲಾಖಾ ಮೌಲ್ಯಮಾಪನ ಸಮಿತಿ ರಚಿಸುವ ಬಗ್ಗೆ.

**ಓದಲಾಗಿದೆ:** 1. ದಿನಾಂಕ 5.6.2003ರ ಯೋಜನೆ, ಸಾಂಖ್ಯಿಕ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ ಇಲಾಖೆಯ ಸುತ್ತೋಲೆ ಸಂಖ್ಯೆ ಯೋಇ 41 ಇವಿ ಎಫ್(1)2003.

2. ದಿ:17.3.2009ರ ಸುತ್ತೋಲೆ ಸಂಖ್ಯೆ: ಪಿಡಿ 4 ಮೌಮಾವಿ 2008.

**ಪ್ರಸ್ತಾವನೆ:**

ಒಂದು ಕೋಟಿ ರೂ.ಗಳಿಗಿಂತ ಹೆಚ್ಚಿನ ಆಯವ್ಯಯ ಹೊಂದಿರುವ ಯೋಜನೆಗಳನ್ನು ಪ್ರತಿ ವರ್ಷ ಮೌಲ್ಯಮಾಪನ ಮಾಡುವ ಸಲುವಾಗಿ ಸರ್ಕಾರದ ಪ್ರಮುಖ ಯೋಜನೆ ಹಾಗೂ ಯೋಜನೇತರ ಕಾರ್ಯಕ್ರಮಗಳನ್ನು ಕಾಲ ಕಾಲಕ್ಕೆ ಮೌಲ್ಯ ಮಾಪನ ಮಾಡುವ ಕುರಿತಂತೆ ಉಲ್ಲೇಖ (1)ರ ಸುತ್ತೋಲೆಯಲ್ಲಿ ಮಾರ್ಗಸೂಚಿಗಳನ್ನು ಹೊರಡಿಸಲಾಗಿದೆ. ಸದರಿ ಮಾರ್ಗಸೂಚಿಗಳನ್ನು ಅನುಬಂಧ 1ರಲ್ಲಿ ನೀಡಲಾಗಿದೆ.

ಉಲ್ಲೇಖ(2)ರ ಸುತ್ತೋಲೆಯಲ್ಲಿ ದಿ:5.6.2003ರ ಸರ್ಕಾರದ ಸುತ್ತೋಲೆಯಂತೆ ಯಾವುದೇ ಇಲಾಖೆಗಳು ಪರಿಷ್ಕೃತ ಮಾರ್ಗಸೂಚಿಗಳನ್ವಯ ಕ್ರಮ ತೆಗೆದುಕೊಳ್ಳದೆ ಇರುವುದರಿಂದ ಇಲಾಖೆಗಳು ವಿಷಯಕ್ಕೆ ಹೆಚ್ಚಿನ ಮಹತ್ವ ನೀಡಿ ಸ್ವತಂತ್ರ ಮೌಲ್ಯಮಾಪನ ಪ್ರಕ್ರಿಯೆಯಲ್ಲಿ ತೊಡಗಿಸಿಕೊಂಡು ಯಾವ ಯಾವ ಯೋಜನೆ/ಕಾರ್ಯಕ್ರಮಗಳನ್ನು ಮೌಲ್ಯಮಾಪನ ಪ್ರಕ್ರಿಯೆಗೆ ಅಳವಡಿಸಿಕೊಳ್ಳಬೇಕೆಂದು ತೀರ್ಮಾನಿಸಿ ಇಲಾಖಾ ಮೌಲ್ಯಮಾಪನ ಸಮಿತಿಯಲ್ಲಿ ಚರ್ಚಿಸಬೇಕೆಂದು ಸೂಚಿಸಿರುವುದರಿಂದ, ಕನ್ನಡ ಮತ್ತು ಸಂಸ್ಕೃತಿ, ವಾರ್ತಾ ಇಲಾಖೆಗೆ ಸಂಬಂಧಿಸಿದಂತೆ ಮೌಲ್ಯಮಾಪನ ಅಧ್ಯಯನಗಳನ್ನು ನಡೆಸುವ ವಿಧಿ ವಿಧಾನಗಳನ್ನೊಳಗೊಂಡಂತೆ ಒಂದು ಇಲಾಖಾ ಮೌಲ್ಯಮಾಪನ ಸಮಿತಿಯನ್ನು ಹಾಗೂ ಆ ಸಮಿತಿಯ ಪ್ರಕಾರ್ಯಗಳನ್ನು ಒಳಗೊಂಡಂತೆ ಆದೇಶವನ್ನು ಹೊರಡಿಸಲು ತೀರ್ಮಾನಿಸಲಾಗಿದೆ. ಆದುದರಿಂದ ಈ ಆದೇಶ.

**ಸರ್ಕಾರದ ಆದೇಶ ಸಂಖ್ಯೆ: ಕಸಂವಾಪ್ರ 87 ಸ್ವೀಮರ 2009, ಬೆಂಗಳೂರು, ದಿ: 20ನೇ ಮೇ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಹಿನ್ನೆಲೆಯಲ್ಲಿ, ಸ್ವತಂತ್ರ ಮೌಲ್ಯಮಾಪನ ಪ್ರಕ್ರಿಯೆಗೆ ಸಂಬಂಧಿಸಿದಂತೆ, ಒಂದು ಕೋಟಿ ರೂ.ಗಳಿಗಿಂತ ಹೆಚ್ಚಿನ ಆಯವ್ಯಯ ಹೊಂದಿರುವ ಯೋಜನೆಗಳನ್ನು ಪ್ರತಿ ವರ್ಷ ಮೌಲ್ಯಮಾಪನ ಮಾಡುವ ಸಲುವಾಗಿ ಸರ್ಕಾರದ ಪ್ರಮುಖ ಯೋಜನೆ ಹಾಗೂ ಯೋಜನೇತರ ಕಾರ್ಯಕ್ರಮಗಳನ್ನು ಕಾಲ ಕಾಲಕ್ಕೆ ಮೌಲ್ಯ ಮಾಪನ ಮಾಡುವ ಕುರಿತಂತೆ ಇಲಾಖೆಗಳು ಹೆಚ್ಚಿನ ಮಹತ್ವ ನೀಡಿ ಸ್ವತಂತ್ರ ಮೌಲ್ಯಮಾಪನ ಪ್ರಕ್ರಿಯೆಯಲ್ಲಿ ತೊಡಗಿಸಿಕೊಳ್ಳಬೇಕಾಗಿರುವುದರಿಂದ ಯಾವ ಯಾವ ಯೋಜನೆ/ಕಾರ್ಯಕ್ರಮಗಳನ್ನು ಮೌಲ್ಯಮಾಪನ ಪ್ರಕ್ರಿಯೆಗೆ ಅಳವಡಿಸಿಕೊಳ್ಳಬೇಕೆಂಬ ಬಗ್ಗೆ ತೀರ್ಮಾನಿಸಲು ಈ ಕೆಳಕಂಡಂತೆ ಇಲಾಖಾ ಮೌಲ್ಯಮಾಪನ ಸಮಿತಿಯನ್ನು ರಚಿಸಲಾಗಿದೆ.

ಇಲಾಖಾ ಮೌಲ್ಯಮಾಪನ ಸಮಿತಿಯು (ಡಿ.ಇ.ಸಿ.) ಈ ಕೆಳಕಂಡಂತಿರುತ್ತದೆ.

| | |
|---|---|
| 1. ಕನ್ನಡ ಮತ್ತು ಸಂಸ್ಕೃತಿ, ವಾರ್ತಾ ಇಲಾಖೆಯ ಕಾರ್ಯದರ್ಶಿಗಳು | – ಅಧ್ಯಕ್ಷರು |
| 2. ಅನುಷ್ಠಾನಗೊಳಿಸುತ್ತಿರುವ ಇಲಾಖೆಯ ಮುಖ್ಯಸ್ಥರುಗಳು | – ಸದಸ್ಯರು |
| 3. ಹಿರಿಯ ನಿರ್ದೇಶಕರು, ಮೌಲ್ಯಮಾಪನ ವಿಭಾಗ ಯೋಜನಾ ಇಲಾಖೆ | – ಸದಸ್ಯರು |
| 4. ಆಂತರಿಕ ಆರ್ಥಿಕ ಸಲಹೆಗಾರರು | – ಸದಸ್ಯರು |
| 5. ಮಾಹಿತಿ ತಂತ್ರಜ್ಞಾನ ಇಲಾಖೆಯ ಪ್ರತಿನಿಧಿ | – ಸದಸ್ಯರು |
| 6. ಸಂಬಂಧಪಟ್ಟ ಇಲಾಖೆಯಲ್ಲಿ ಯೋಜನೆ ಮತ್ತು ಮಾನಿಟರಿಂಗ್ ಕಾರ್ಯ ನಿರ್ವಹಿಸುತ್ತಿರುವ ಉಪ ಕಾರ್ಯದರ್ಶಿಗಳು | – ಸದಸ್ಯ–ಕಾರ್ಯದರ್ಶಿಗಳು |

**ಸಮಿತಿಯ ಪ್ರಕಾರ್ಯಗಳು ಕೆಳಗಿನಂತಿವೆ:**

1. ಮೌಲ್ಯಮಾಪನಕ್ಕೆ ಒಳಪಡಿಸಬೇಕಾದ ಯೋಜನೆ/ಕಾರ್ಯಕ್ರಮಗಳ ಬಗ್ಗೆ ನಿರ್ಧರಿಸುವುದು.
2. ಮೌಲ್ಯಮಾಪನವನ್ನು ಹೊರಗಿನ ಸಂಸ್ಥೆಗಳಿಗೆ ವಹಿಸುವುದು
3. ಮೌಲ್ಯಮಾಪನ ಸಂಸ್ಥೆಗಳು ತಯಾರಿಸಿದ ಮೌಲ್ಯಮಾಪನ ವರದಿಗಳನ್ನು ಪರಿಶೀಲಿಸಿ ಅಂತಿಮಗೊಳಿಸುವುದು
4. ಮೌಲ್ಯಮಾಪನ ಅಧ್ಯಯನದಲ್ಲಿನ ಶಿಫಾರಸ್ಸುಗಳನ್ನು ಅಂತಿಮಗೊಳಿಸುವುದು ಹಾಗೂ ಶಿಫಾರಸ್ಸುಗಳ ಮೇಲಿನ ಅನುವರ್ತನಾ ಕ್ರಮಗಳನ್ನು ಸೂಚುಸುವುದು.
5. ಮೇಲಿನ 4ರಲ್ಲಿ ಅಂತಿಮಗೊಳಿಸಿದ ಅನುವರ್ತನಾ ಕ್ರಮಗಳ ಅನುಷ್ಠಾನದ ಪರಿಶೀಲನೆ.

ಮೌಲ್ಯಮಾಪನ ಪ್ರಕ್ರಿಯೆಗೆ ಅಳವಡಿಸುವ ಯೋಜನೆಗಳು ಕನಿಷ್ಠ 2–3 ವರ್ಷಗಳಿಂದ ಅನುಷ್ಠಾನದಲ್ಲಿರಬೇಕು ಮತ್ತು 2009–10ನೇ ಸಾಲಿನಲ್ಲಿ ಅದು ಮುಂದುವರೆದ ಯೋಜನೆಯಾಗಿರತಕ್ಕದ್ದು. ಹಾಗೂ ಇಲಾಖೆಗಳು ಮೌಲ್ಯಮಾಪನ ಯೋಜನೆಗಳನ್ನು ಆಯ್ಕೆ ಮಾಡಿದ ನಂತರ ದಿ:5.6.2003ರ ಸುತ್ತೋಲೆಯ ಪ್ಯಾರಾ–6ರಲ್ಲಿ ಸೂಚಿಸಿರುವಂತೆ ಕರಡು ಸಂಕ್ಷಿಪ್ತ ಪರಿಕಲ್ಪನಾ ಬರಹವನ್ನು ಈ ಕೆಳಕಂಡ ವಿಷಯಗಳನ್ನೊಳಗೊಂಡಿರುವಂತೆ ತಯಾರಿಸತಕ್ಕದ್ದು.

1. ಮೌಲ್ಯಮಾಪನಕ್ಕೆ ಈ ಯೋಜನೆಯನ್ನು ಏಕೆ ಆಯ್ಕೆ ಮಾಡಲಾಗಿದೆ
2. ಮೌಲ್ಯಮಾಪನದಿಂದ ಏನನ್ನು ತಿಳಿಯಲು ಬಯಸಲಾಗಿದೆ(ಮೌಲ್ಯಮಾಪನದ ಉದ್ದೇಶ ಮತ್ತು ಅಳತೆ ಗೋಲುಗಳನ್ನು ವಿವರಿಸುವುದು)
3. ಮೌಲ್ಯ ಮಾಪನದ ವಿನ್ಯಾಸ ಉದಾ: ಸಮೀಕ್ಷೆ/ವಿಷಯ ಅಧ್ಯಯನ (Case study)ಮುಂತಾದವು.
4. ಸಂಬಂಧಪಟ್ಟ ಇಲಾಖೆಗಳು ಮೌಲ್ಯಮಾಪನದ ಫಲಿತಾಂಶವನ್ನು ಹೇಗೆ ಉಪಯೋಗಿಸಿಕೊಳ್ಳುತ್ತವೆ.

ಮೇಲಿನ ಅಂಶಗಳಲ್ಲದೆ ಮೌಲ್ಯಮಾಪನ ಪ್ರಕ್ರಿಯೆಗೆ ಸಂಬಂಧಿಸಿದಂತೆ ಯೋಜನಾ ಇಲಾಖೆಯು ದಿನಾಂಕ 5.6.2003ರಂದು ಹೊರಡಿಸಿರುವ ಪರಿಷ್ಕೃತ ಮಾರ್ಗಸೂಚಿಗಳನ್ವಯ ಸಮಿತಿಯು ಕಾರ್ಯನಿರ್ವಹಿಸತಕ್ಕದ್ದು. ಆ ಮಾರ್ಗಸೂಚಿಗಳನ್ನು ಅನುಬಂಧ –1ರಲ್ಲಿ ನೀಡಲಾಗಿದೆ.

**ಇಲಾಖಾ ಮೌಲ್ಯಮಾಪನ ಸಮಿತಿಯು ಈ ಕೆಳಕಂಡಂತ ವೇಳಾಪಟ್ಟಿಯನ್ವಯ ಕಾರ್ಯನಿರ್ವಹಿಸತಕ್ಕದ್ದು.**

| (1) | (2) | (3) | (4) |
|---|---|---|---|
| ಮೌಲ್ಯಮಾಪನ ಅಧ್ಯಯನಕ್ಕೆ ವಿಷಯವನ್ನು ಆಯ್ಕೆ ಮಾಡುವುದು, ಸಲಹೆಗಾರರ ಪೂರ್ವಾರ್ಹತೆ ಕಿರುಪಟ್ಟಿ ಮತ್ತು ಷರತ್ತುಗಳನ್ನು ಅನುಮೋದಿಸಲು ಇಲಾಖಾ ಮೌಲ್ಯಮಾಪನ ಸಮಿತಿ ಸಭೆ (ಏಪ್ರಿಲ್) | ಮೌಲ್ಯಮಾಪನ ಅಧ್ಯಯನ ವರದಿಗಳನ್ನು ಅನುಮೋದಿಸಲು ಇಲಾಖಾ ಮೌಲ್ಯಮಾಪನ ಸಮಿತಿ ಸಭೆ (ಆಗಸ್ಟ್–ಸೆಪ್ಟೆಂಬರ್) | ಅಧ್ಯಯನ ವರದಿಯ ಶಿಫಾರಸ್ಸುಗಳ ಮೇಲೆ ಕ್ರಮ ಕೈಗೊಳ್ಳಲು ಅಂಶಗಳನ್ನು ನಿರ್ಧರಿಸಲು ಹಾಗೂ ಸಾಧ್ಯವಿರುವೆಡೆ ಯೋಜನೆಯ ಜಾರಿಯಲ್ಲಿ ಮಧ್ಯಂತರ ತಿದ್ದಪಡಿಗಳನ್ನು ಸೂಚಿಸುವುದು (ಅಕ್ಟೋಬರ್–ಡಿಸೆಂಬರ್) | ಶಿಫಾರಸ್ಸುಗಳ ಸಾರಾಂಶ ಮತ್ತು ಕ್ರಮ ತೆಗೆದುಕೊಂಡ ವರದಿಯನ್ನು ಮೌಲ್ಯಮಾಪನ ಸಮನ್ವಯ (ಇಸಿಸಿ)ಸಮಿತಿಯ ಮುಂದಿರಿಸುವುದು. (ಡಿಸೆಂಬರ್–ಮಾರ್ಚ್) |

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಎಂ.ಕೆ. ಭರ್ಮರಾಜಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ,

ಕನ್ನಡ ಮತ್ತು ಸಂಸ್ಕೃತಿ, ವಾರ್ತಾ ಮತ್ತು ಪ್ರವಾಸೋದ್ಯಮ ಇಲಾಖೆ.

## ANNEXURE – I

### Revised Guidelines for independent evaluation initiative

1. To initiate evaluation, one major plan/non-plan scheme has to be selected.
2. It should be done by an independent agency.
3. No special finance will, be provided for the same by Planning Department.
4. The department can take up different types of evaluations like impact monitoring, process evaluation and impact evaluation.
5. The Administrative Departments should ask the field departments to initiate evaluation and submit at least one evaluation report within 31st March of every year.
6. A department which intends to outsource the Evaluation study to an external agency should prepare a draft concept paper summarizing-
   a. Why the scheme is being picked for Evaluation.
   b. What is hoped will be learnt from the Evaluation (defining the parameters and objectives of the evaluation).
   c. How it is planned that this will be learnt (evaluation design e.g. survey/case study etc.,)
   d. How the information will be used by the department concerned.
7. Pre-qualifying criteria for short-listing consultants.
   a. The department can circulate the concept paper among the consultants (list of addresses provided by the Planning Department) and ask for their expression of interest.
   b. The concept paper should be sent to those consultant who are specialized in a particular area.
   c. An advertisement inviting offers from the interested agencies may be published in selected newspapers giving 3 weeks time for submission of proposals form the date of publication.
   d. The agency can be selected on the basis of a comparative statement of offers prepared by the Department.
   e. Particulars of the selected agencies may be obtained through direct communication with them.
   f. The agency can be selected on the basis of comparative merits of the agencies.
   g. A single agency can also be selected, provided such an agency is having good reputation, experience in conducting studies and best suited for the study proposed.

8. Utilizing the concept paper, the Terms of Reference will be drafted and an agreement (with the agency) entered into.
9. Once the evaluation questions are decided as mentioned in 7(b) & 7(c), by looking at the evaluation design the Department can ask the agency to conduct the evaluation study at per the design.
10. As far as possible, the department must integrate gender issues in the evaluation questions and design.
11. A draft report will be submitted by the agency within the stipulated time to the department concerned. The department in turn before making final payment should satisfy itself that all the issues mentioned in the TOR have been covered.
12. If the draft report submitted by the external agency is unsatisfactory with regard to the TOR then the department may impose a penalty and this should be mentioned in the TOR.
13. Draft reports submitted by the agencies will be discussed in the DEC.A separate meeting need not be called for this. The MMR can be a forum for such discussions. In that case, only the other two members namely, Senior Director, Evaluation Division of Planning Department and the representative of Directorate of IT who are the members of the DEC have to be invited for the meeting. Further, the services of the Nodal Officers of the Planning Department may be utilized for the purpose.
14. Each such meeting should invariably have proceedings for follow- up actions.
15. The department which has outsourced the study should prepare a one page summary of the report and present the findings and recommendations of the study in the DEC meeting. The Committee can finalize the recommendations, approve the report and suggest actions on the recommendations. The one page summary of the report should be sent to the Evaluation Division through a Floppy so as to enable the Planning Department to corporate the abstract in the Evaluation Database.
16. The Committee should take follow-up action on the recommendations so that the report and the Action Taken Report (ATR) could be placed before the ECC for its approval. The ATR should be sent to the planning Department within 2 months after the DEC meeting.
17. The Department should forward Two hard copies and a soft copy (CD) of the report to the Senior Director, Evaluation Division, Planning, Statistics, Science & Technology Department, 6th floor, II stage, M.S. Building in order to submit to the ECC and put the same on the website of the planning Department. The soft copy should be prepared in Portable Document Format (PDF) with a file name, and links to all the chapters of the report, through index.
18. The agencies should prepare the report with the following contents; executive summary, the TOR, the questionnaire used, the statistical tools used, background notes and a separate chapter on findings and recommendations.
19. The Departments should send the Quarterly Progress Report (QPR) to the Planning Department, within a week after the end of the quarter.
20. The above mentioned are only broad guidelines. Departments can select any scheme either plan or non-plan- if it is significant, even if the allocation for the scheme is less than Rs. 1 crore.

**ಎಂ.ಕೆ. ಧರ್ಮರಾಜಪ್ಪ**
ಪಿ.ಆರ್. 1311 ಸರ್ಕಾರದ ಅಧೀನ ಕಾರ್ಯದರ್ಶಿ,
ಕನ್ನಡ ಮತ್ತು ಸಂಸ್ಕೃತಿ, ವಾರ್ತಾ ಮತ್ತು ಪ್ರವಾಸೋದ್ಯಮ ಇಲಾಖೆ.

## ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಸಚಿವಾಲಯ

**ವಿಷಯ:** ಕರ್ನಾಟಕ ರಾಜ್ಯ ಮಹಿಳಾ ಆಯೋಗಕ್ಕೆ ವೃಂದ ಮತ್ತು ನೇಮಕಾತಿ ನಿಯಮಗಳನ್ನು ರಚಿಸಲು ಉಪಸಮಿತಿಯನ್ನು ರಚಿಸುವ ಬಗ್ಗೆ.

**ಓದಲಾಗಿದೆ:** ಕಾರ್ಯದರ್ಶಿಗಳು, ಕರ್ನಾಟಕ ರಾಜ್ಯ ಮಹಿಳಾ ಆಯೋಗ, ಬೆಂಗಳೂರು ರವರ ಕಛೇರಿಯ ಏಕ ಕಡತ ಸಂಖ್ಯೆ:ಕರಾಮಆ/ಏಕ ಕಡತ–/2009–10 ದಿನಾಂಕ: 05.05.2009.

**ಪ್ರಸ್ತಾವನೆ:**

ಮೇಲೆ ಓದಲಾದ ದಿನಾಂಕ:05.05.2009ರ ಏಕ ಕಡತದ ಟಿಪ್ಪಣಿಯಲ್ಲಿ ಕಾರ್ಯದರ್ಶಿಗಳು, ಕರ್ನಾಟಕ ರಾಜ್ಯ ಮಹಿಳಾ ಆಯೋಗ, ಬೆಂಗಳೂರು ರವರು ಕರ್ನಾಟಕ ರಾಜ್ಯ ಮಹಿಳಾ ಆಯೋಗದ ವೃಂದ ಮತ್ತು ನೇಮಕಾತಿ ನಿಯಮಗಳನ್ನು ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಇಲಾಖೆಯ ಅಧ್ಯಕ್ಷತೆಯಲ್ಲಿ ಉಪಸಮಿತಿಯನ್ನು ರಚಿಸುವಂತೆ ಕೋರಿರುತ್ತಾರೆ.

ಕಾರ್ಯದರ್ಶಿಗಳು, ಕರ್ನಾಟಕ ರಾಜ್ಯ ಮಹಿಳಾ ಆಯೋಗದ ಪ್ರಸ್ತಾವನೆಯನ್ನು ಪರಿಶೀಲಿಸಿ, ನಿರ್ದೇಶಕರು, ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಇಲಾಖೆ, ಇವರ ಅಧ್ಯಕ್ಷತೆಯಲ್ಲಿ ವೃಂದ ಮತ್ತು ನೇಮಕಾತಿ ನಿಯಮಗಳ ಉಪಸಮಿತಿಯೊಂದನ್ನು ರಚಿಸಲು ತೀರ್ಮಾನಿಸಿ ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಮಮಇ 237 ಎಸ್‌ಜಿಡಿ 2009, ಬೆಂಗಳೂರು, ದಿನಾಂಕ: 12ನೇ ಮೇ 2009**

ಕರ್ನಾಟಕ ರಾಜ್ಯ ಮಹಿಳಾ ಆಯೋಗದ ವೃಂದ ಮತ್ತು ನೇಮಕಾತಿ ನಿಯಮಗಳನ್ನು ರಚಿಸಲು ಈ ಕೆಳಕಂಡ ಉಪಸಮಿತಿಯನ್ನು ತಕ್ಷಣದಿಂದ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆಗೆ ರಚಿಸಿದೆ.

| | | | |
|---|---|---|---|
| 1 | ನಿರ್ದೇಶಕರು<br>ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಇಲಾಖೆ | – | ಅಧ್ಯಕ್ಷರು |
| 2 | ಸರ್ಕಾರದ ಅಪರ ಕಾರ್ಯದರ್ಶಿ,<br>ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆ | – | ಸದಸ್ಯರು |
| 3 | ಸರ್ಕಾರದ ಉಪಕಾರ್ಯದರ್ಶಿ,<br>ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಇಲಾಖೆ | – | ಸದಸ್ಯರು |
| 4 | ಸರ್ಕಾರದ ಉಪಕಾರ್ಯದರ್ಶಿ,<br>ಆರ್ಥಿಕ ಇಲಾಖೆ (ಸೇವೆಗಳು) | – | ಸದಸ್ಯರು |
| 5 | ಸರ್ಕಾರದ ಅಧೀನ ಕಾರ್ಯದರ್ಶಿ,<br>ಸಿ.ಆ.ಸು.ಇ (ಸೇವಾ ನಿಯಮಗಳು–3) | – | ಸದಸ್ಯರು |
| 6 | ಕಾರ್ಯದರ್ಶಿಗಳು,<br>ಕರ್ನಾಟಕ ರಾಜ್ಯ ಮಹಿಳಾ ಆಯೋಗ | – | ಸದಸ್ಯ ಕಾರ್ಯದರ್ಶಿ |

ಸದರಿ ಸಮಿತಿಯು 2 ತಿಂಗಳ ಅವಧಿಯಲ್ಲಿ ಕರಡು ನಿಯಮಗಳನ್ನು ರಚಿಸಲು ಸೂಚಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಆರ್. ನರಸಿಂಹಯ್ಯ**

ಪಿ.ಆರ್. 1312

ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರ),
ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಇಲಾಖೆ.

## ಒಳಾಡಳಿತ ಸಚಿವಾಲಯ

**ವಿಷಯ:** ಪೊಲೀಸ್ ಆಧುನೀಕರಣ ಕ್ರಿಯಾ ಯೋಜನೆಯಡಿಯಲ್ಲಿ ಅನುದಾನ ಬಿಡುಗಡೆ ಮಾಡುವ ಬಗ್ಗೆ.

**ಓದಲಾಗಿದೆ:** 1. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರವರ ಪತ್ರ ಸಂಖ್ಯೆ:1/ಎಡಿಜಿಪಿ/ಟಿಟಿಎಂ/2009–10, ದಿನಾಂಕ:09.04.2009.

2. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರವರ ಪತ್ರ ಸಂಖ್ಯೆ:1/ಎಡಿಜಿಪಿ/ಟಿಟಿಎಂ/Suppl.Plan(Part-B)08–09, ದಿನಾಂಕ:09.04.2009.

**ಪ್ರಸ್ತಾವನೆ:**

1. ಮೇಲೆ ಓದಲಾದ ಕ್ರಮ ಸಂಖ್ಯೆ (1)ರಲ್ಲಿ ದಿನಾಂಕ:09.04.2009ರ ಪತ್ರದಲ್ಲಿ ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು ರವರ ಸರ್ಕಾರಕ್ಕೆ ಪ್ರಸ್ತಾವನೆಯನ್ನು ಸಲ್ಲಿಸಿ, ಪೊಲೀಸ್ ಆಧುನೀಕರಣ ಯೋಜನೆಯಡಿಯಲ್ಲಿ ಕರ್ನಾಟಕ ರಾಜ್ಯಕ್ಕೆ 2008–09ನೇ ಸಾಲಿಗೆ ಕೇಂದ್ರ ಸರ್ಕಾರದಿಂದ ಬಿಡುಗಡೆ ಮಾಡಲಾದ ಅನುದಾನ ರೂ.3,02,78,897/–ಗಳನ್ನು ಬೆಂಗಳೂರು ನಗರಕ್ಕೆ ಡಿಜಿಟೇಲ್ ರೇಡಿಯೋ ಟ್ರಂಕಿಂಗ್ ಸಿಸ್ಟಮ್ (Digital Radio Trunking System) ನ್ನು ಅಳವಡಿಸಲು ಮೀಸಲಾಗಿರುವುದರಿಂದ ಸದರಿ ಅನುದಾನವನ್ನು ಡಿಜಿ ಮತ್ತು ಐಜಿಪಿ ರವರಿಗೆ ಬಿಡುಗಡೆ ಮಾಡಿ ತದನಂತರ ಸದರಿ ಅನುದಾನವನ್ನು ಬೆಂಗಳೂರು ನಗರಕ್ಕೆ ಡಿಜಿಟೇಲ್ ರೇಡಿಯೋ ಟ್ರಂಕಿಂಗ್ ಸಿಸ್ಟಮ್ (Digital Radio Trunking System) ನ್ನು ಅಳವಡಿಸಲು ಪೇಯೀಸ್ ರಸೀಟ್ (Payees Receipt) ಮೇಲೆ ಡ್ರಾ ಮಾಡಿ ಮೆ॥ ಕರ್ನಾಟಕ ರಾಜ್ಯ ಗೃಹ ನಿರ್ಮಾಣ ನಿಗಮ ನಿಯಮಿತ, ಬೆಂಗಳೂರು ರವರ ಖಾತೆಯಲ್ಲಿ ಠೇವಣಿ ಇಡಲು ಸರ್ಕಾರದ ಮಂಜೂರಾತಿಯನ್ನು ಕೋರಿರುತ್ತಾರೆ.

2. ಮೇಲೆ ಓದಲಾದ ಕ್ರಮ ಸಂಖ್ಯೆ (2)ರಲ್ಲಿ ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು ರವರು ಸರ್ಕಾರಕ್ಕೆ ಪ್ರಸ್ತಾವನೆಯನ್ನು ಸಲ್ಲಿಸಿ, ಪೊಲೀಸ್ ಆಧುನೀಕರಣ ಯೋಜನೆಯಡಿಯಲ್ಲಿ ಕರ್ನಾಟಕ ರಾಜ್ಯಕ್ಕೆ 2008–09ನೇ ಸಾಲಿಗೆ ಕೇಂದ್ರ ಸರ್ಕಾರದಿಂದ ಬಿಡುಗಡೆ ಮಾಡಲಾದ ಅನುದಾನ ರೂ.9,81,50,163/– ಗಳನ್ನು ಅನುಮೋದನೆಗೊಂಡ ಯೋಜನೆಗಳಿಗೆ ಉಪಯೋಗಿಸಿಕೊಳ್ಳಲು ಮಂಜೂರು ಮಾಡುವ ಬಗ್ಗೆ ಕೋರಿರುತ್ತಾರೆ.

ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು ರವರ ಪ್ರಸ್ತಾವನೆಗಳನ್ನು ಪರಿಶೀಲಿಸಿ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ:ಹೆಚ್‌ಡಿ:11:ಪಿಎಫ್‌ಎಸ್:2007, ಬೆಂಗಳೂರು, ದಿನಾಂಕ: 23ನೇ ಮೇ 2009**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ, 2009–10ನೇ ಸಾಲಿನ ಆಯವ್ಯಯದಲ್ಲಿ Modernisation of Police Force's ಗೆ ಲೆಕ್ಕ ಶೀರ್ಷಿಕೆ 2055–00–115–0–00 (ಯೋಜನೇತರ) ರಡಿ ರೂ.9826.81 ಲಕ್ಷ ಒದಗಿಸಿದ್ದು ಇದರಡಿ ಕೇಂದ್ರದಿಂದ ಈಗಾಗಲೇ ಜಮೆಯಾಗಿರುವ ರೂ.3,02,78,897 + 9,81,50,163 ಅಂದರೆ ಒಟ್ಟು ರೂ.12,84,29,060/–ಗಳನ್ನು (ಹನ್ನೆರಡು ಕೋಟಿ ಎಂಬತ್ನಾಲ್ಕು ಲಕ್ಷ ಇಪ್ಪತ್ತೊಂಭತ್ತು ಸಾವಿರದ ಅರವತ್ತು ರೂಪಾಯಿಗಳು ಮಾತ್ರ) ಬಿಡುಗಡೆ ಮಾಡಲಾಗಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆ:ಆಇ:444:ವೆಚ್ಚ–11:2009 ದಿನಾಂಕ:13/05/2009ರ ಸಹಮತಿಯ ಮೇರೆಗೆ ಹೊರಡಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1313

**ಬಿ.ಎಂ. ಲಕ್ಷ್ಮೀನಾರಾಯಣ**

ಸರ್ಕಾರದ ಅಧೀನ ಕಾರ್ಯದರ್ಶಿ, ಒಳಾಡಳಿತ ಇಲಾಖೆ. (ಪೊಲೀಸ್ ವೆಚ್ಚ)

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ಮರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಕನ್ನಾಳ ಗ್ರಾಮದ ಜಮೀನುಗಳಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಐತೀರ್ಪಿನಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 21/02/2009ರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಭೂಸ್ವಾ/2008–09/1203.

**ಪ್ರಸ್ತಾವನೆ:**

ಮೇಲೆ ಓದಲಾದ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ದಿನಾಂಕ 21/02/09ರ ಪತ್ರದಲ್ಲಿ ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ಮರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಕನ್ನಾಳ ಗ್ರಾಮದ ಜಮೀನುಗಳಿಗೆ ಕೊಪ್ಪಳದ ಉಪ ವಿಭಾಗಾಧಿಕಾರಿಗಳು ಭೂಸ್ವಾಧೀನ ಕಾಯ್ದೆ ಕಲಂ 28(ಎ)ರ ಪ್ರಕಾರ ಉಪ ವಿಭಾಗಾಧಿಕಾರಿಗಳು ಹಾಗೂ ಭೂಸ್ವಾಧೀನಾಧಿಕಾರಿಗಳು, ಕೊಪ್ಪಳ ಇವರು ಹೊರಡಿಸಿದ ಐತೀರ್ಪಿನಂತೆ ಪರಿಹಾರ ಧನ ಪಾವತಿಸಲು ರೂ.21,87,667–00ಗಳನ್ನು ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಈ ಕೆರೆಯ ಮೂಲ ಭೂಸ್ವಾಧೀನ ಪ್ರಕ್ರಿಯೆಯ ವಿವರಗಳು ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 29/03/2001
- ಉಪ ವಿಭಾಗಾಧಿಕಾರಿಗಳ ಐತೀರ್ಪಿನ ದಿನಾಂಕ 15/03/2003

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕಿನ ಮರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಕನ್ನಾಳ ಗ್ರಾಮದ ಸ.ನಂ.24/3,4,5,6 ರ 7–25 ಎಕರೆ ಜಮೀನಿಗೆ ಕೊಪ್ಪಳ ಉಪವಿಭಾಗಾಧಿಕಾರಿಗಳು ಹಾಗೂ ಭೂಸ್ವಾಧೀನಾಧಿಕಾರಿಗಳು ಎಲ್.ಎ.ಸಿ. ಸಂಖ್ಯೆ:59/05ರಲ್ಲಿ ನೀಡಿದ ತೀರ್ಪನ್ನು ಉಲ್ಲೇಖಿಸಿ ಈ ಭೂಸ್ವಾಧೀನ ಪ್ರಕ್ರಿಯೆಯಲ್ಲಿ ಸೇರಿದ್ದ ಇತರೆ ಸ.ನಂ.ಗಳ ಜಮೀನಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ಹೊರಡಿಸಿರುವ ಐತೀರ್ಪಿನಂತೆ ಪಾವತಿಸಬೇಕಾದ ಪರಿಹಾರ ಧನದ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ. ಸಂ | ಕನ್ನಾಳ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ. | ಭೂ.ಸ್ವಾ. ಕಾಯ್ದೆ ಕಲಂ 28(ಎ)ರಡಿ ಐತೀರ್ಪಿನ ಸಂಖ್ಯೆ ಮತ್ತು ದಿನಾಂಕ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 24/3, 4, 5, 6 | 7–25 | ಕಂ/ಭೂಸ್ವಾ/ಸಾ/14/2000–01/28(ಎ)/ಅಪೀಲು ದಿನಾಂಕ 30/08/08 | 21,87,667–00 |

ವಿಷಯವನ್ನು ಪರಿಶೀಲಿಸಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 53 ಭೂಸ್ವಾಪ್ರ 2009, ಬೆಂಗಳೂರು, ದಿನಾಂಕ: 22ನೇ ಮೇ 2009.**

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕು ಮರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಕನ್ನಾಳ ಗ್ರಾಮದ ಜಮೀನುಗಳಿಗೆ ಕೊಪ್ಪಳದ ಉಪ ವಿಭಾಗಾಧಿಕಾರಿಗಳು ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ಉಪ

ವಿಭಾಗಾಧಿಕಾರಿಗಳು, ಕೊಪ್ಪಳ ಇವರು ದಿನಾಂಕ 30/08/2008ರಂದು ಹೊರಡಿಸಿದ ಐತೀರ್ಪಿನಂತೆ ಪರಿಹಾರ ಧನದ ಮೊತ್ತ ರೂ.21,87,667–00ಗಳನ್ನು (ಇಪ್ಪತ್ತೊಂದು ಲಕ್ಷದ ಎಂಭತ್ತೇಳು ಸಾವಿರದ ಆರುನೂರ ಅರವತ್ತೇಳು ರೂ.ಗಳು ಮಾತ್ರ) ಪ್ರಸ್ತಾವನೆಯಲ್ಲಿ ತಿಳಿಸಿರುವ ಸ.ನಂ.ನ ಜಮೀನಿಗೆ ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

ಈ ವೆಚ್ಚವನ್ನು 2009–10ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಕೂಡಲೇ ಸಂಬಂಧಿಸಿದ ಸಣ್ಣ ನೀರಾವರಿ ಅಧಿಕಾರಿಗಳು ವರ್ಗಾವಣೆ ಬಗ್ಗೆ ಕ್ರಮ ಕೈಗೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2008, ದಿನಾಂಕ 16/05/2008ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1321

**ಕೆ. ಸುಧಾಕರ ಶೆಟ್ಟಿ**

ಸರ್ಕಾರದ ಅಧೀನ ಕಾರ್ಯದರ್ಶಿ, ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ)

## ಇಂಧನ ಸಚಿವಾಲಯ

**ವಿಷಯ:** ಮೆ:: Chamundeshwari Energy Pvt. Ltd. ಕಂಪನಿಗೆ 3.00 ಮೆಗಾ ವ್ಯಾಟ್ ಸಾಮರ್ಥ್ಯದ ಹಲ್ಲಿಹೊಳೆ ಕಿರು ಜಲ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡುವ ಬಗ್ಗೆ.

**ಓದಲಾಗಿದೆ:** 1 ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತ ಸಂಸ್ಥೆಯ ವ್ಯವಸ್ಥಾಪಕ ನಿರ್ದೇಶಕರ ಪತ್ರ ಸಂಖ್ಯೆ: ಕೆಆರ್‌ಇಡಿ/06/ಹಲ್ಲಿಹೊಳೆ/07/2967 ದಿನಾಂಕ: 24/25.01.2008.

2 ದಿನಾಂಕ: 13.2.2009 ರಂದು ನಡೆದ ಹಂಚಿಕೆ ಸಮಿತಿ ಸಭೆಯ ನಡವಳಿಗಳು.

**ಪ್ರಸ್ತಾವನೆ :–**

ಮೇಲೆ ಓದಲಾದ ಕ್ರಮ ಸಂಖ್ಯೆ (1) ರ ಪತ್ರದಲ್ಲಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ವ್ಯವಸ್ಥಾಪಕ ನಿರ್ದೇಶಕರು ಮೆ:: Chamundeshwari Energy Pvt. Ltd. ಕಂಪನಿಗೆ ಉಡುಪಿ ಜಿಲ್ಲೆಯ ಕುಂದಾಪುರ ತಾಲ್ಲೂಕಿನ ಹಲ್ಲಿಹೊಳೆ ಗ್ರಾಮದ ಬಳಿ ಚಕ್ರಾ ನದಿಗೆ ಅಡ್ಡಲಾಗಿ 3.00 ಮೆಗಾ ವ್ಯಾಟ್ ಸಾಮರ್ಥ್ಯದ ಹಲ್ಲಿಹೊಳೆ ಕಿರು ಜಲ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡುವಂತೆ ಸರ್ಕಾರಕ್ಕೆ ಶಿಫಾರಸ್ಸು ಮಾಡಿರುತ್ತಾರೆ.

ಮೇಲೆ ಓದಲಾದ ಕ್ರಮ ಸಂಖ್ಯೆ (2) ರ ಹಂಚಿಕೆ ಸಮಿತಿ ಸಭೆಯಲ್ಲಿ ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಅನುಮೋದನೆ ನೀಡಲಾಗಿದೆ. ಆದುದರಿಂದ, ಈ ಕೆಳಗಿನಂತೆ ಆದೇಶಿಸಲಾಗಿದೆ :–

**ಸರ್ಕಾರದ ಆದೇಶ ಸಂಖ್ಯೆ: ಇಎನ್ 46 ಎನ್‌ಸಿಇ 2008, ಬೆಂಗಳೂರು, ದಿನಾಂಕ: 19ನೇ ಮೇ 2009.**

ಮೆ:: Chamundeshwari Energy Pvt. Ltd. ಕಂಪನಿಗೆ ಉಡುಪಿ ಜಿಲ್ಲೆಯ ಕುಂದಾಪುರ ತಾಲ್ಲೂಕಿನ ಹಲ್ಲಿಹೊಳೆ ಗ್ರಾಮದ ಬಳಿ ಚಕ್ರಾ ನದಿಗೆ ಅಡ್ಡಲಾಗಿ 3.00 ಮೆಗಾ ವ್ಯಾಟ್ ಸಾಮರ್ಥ್ಯದ ಹಲ್ಲಿಹೊಳೆ ಕಿರು ಜಲ ವಿದ್ಯುತ್ ಯೋಜನೆಯನ್ನು (**Latitude**: 13 44'30", **Longitude**: 74 54'18")

ಈ ಕೆಳಗಿನ ನಿಬಂಧನೆಗೊಳಪಟ್ಟು ಹಂಚಿಕೆ ಮಾಡಲಾಗಿದೆ:–

1(ಅ) ಸದರಿ ಯೋಜನೆಯಿಂದ ಕೆಳ ತೊರೆ ಮತ್ತು ಮೇಲ್ತೊರೆ ಯೋಜನೆಗಳಿಗೆ ಯಾವುದೇ ಹಾನಿಯಾಗಬಾರದು.

(ಆ) ಹಂಚಿಕೆದಾರರು ಈ ಆದೇಶ ಹೊರಡಿಸಿದ ಮೂರು ತಿಂಗಳ ಒಳಗಾಗಿ ಸರ್ಕಾರದೊಂದಿಗೆ ಒಡಂಬಡಿಕೆಯನ್ನು ಮಾಡಿಕೊಳ್ಳತಕ್ಕದ್ದು. ಇಲ್ಲದಿದ್ದಲ್ಲಿ, ಈ ಹಂಚಿಕೆ ತಂತಾನೇ ರದ್ದಾಗುವುದು. ನಂತರ, ಕಂಪನಿಯು ಹಂಚಿಕೆಗೋಸ್ಕರ ಪುನಃ ಹೊಸದಾಗಿ ಅರ್ಜಿ ಸಲ್ಲಿಸತಕ್ಕದ್ದು. ಯಾವ ಕಾರಣಕ್ಕೂ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತವು ಸ್ವೀಕರಿಸಿದ ಅರ್ಜಿ ಪರಿಷ್ಕರಣಾ ಶುಲ್ಕವನ್ನು ಹಿಂದಿರುಗಿಸಲಾಗುವುದಿಲ್ಲ.

(ಇ) ಒಡಂಬಡಿಕೆಯನ್ನು ರೂ. 400.00ರ ಛಾಪಾ ಕಾಗದದ ಮೇಲೆ ಮಾಡಿಕೊಂಡು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದವರಿಗೆ ಕಳುಹಿಸಿ ಪ್ರಮಾಣೀಕರಿಸಿ ಸರ್ಕಾರಕ್ಕೆ ಕಳುಹಿಸಿಕೊಡತಕ್ಕದ್ದು.

(ಈ) ಈ ಒಡಂಬಡಿಕೆಯನ್ನು ಮಾಡಿಕೊಳ್ಳುವ ಮೊದಲು ಯೋಜನಾ ಅಭಿವೃದ್ಧಿದಾರರು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮತಕ್ಕೆ ವಿವರವಾದ ಯೋಜನಾ ವರದಿಯನ್ನು (ಡಿ.ಪಿ.ಆರ್) ಪರಿಷ್ಕರಿಸಲು ಮೆಗಾವಾಟ್ ಒಂದಕ್ಕೆ ರೂ. 25,000.00 ದಂತೆ ರೂ. 1.00 ಲಕ್ಷಕ್ಕೆ ಕಡಿಮೆ ಇಲ್ಲದಂತೆ ಪಾವತಿಸತಕ್ಕದ್ದು.

2(ಅ) ಯೋಜನಾ ಅಭಿವೃದ್ಧಿದಾರರು ಸಂಬಂಧಪಟ್ಟ ಎಲ್ಲಾ ಇಲಾಖೆಗಳಿಂದಲೂ ಅಂದರೆ ಜಲಸಂಪನ್ಮೂಲ ಇಲಾಖೆ, ಅರಣ್ಯ, ಜೀವಿಶಾಸ್ತ್ರ & ಪರಿಸರ ಇಲಾಖೆ, ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತ, ಕರ್ನಾಟಕ ವಿದ್ಯುತ್ ನಿಗಮ ನಿಯಮಿತ, ಕರ್ನಾಟಕ ಮಾಲಿನ್ಯ ನಿಯಂತ್ರಣ ಮಂಡಳಿ ಮತ್ತು ಕಂದಾಯ ಇಲಾಖೆಗಳಿಂದ ಕ್ಲಿಯರೆನ್ಸ್‌ಗಾಗಿ ಅರ್ಜಿ ಸಲ್ಲಿಸತಕ್ಕದ್ದು. ಒಡಂಬಡಿಕೆ ಮಾಡಿಕೊಂಡ ಒಂದು ವರ್ಷದೊಳಗಾಗಿ ವಿವರವಾದ ಯೋಜನಾ ವರದಿಯನ್ನು ಸಲ್ಲಿಸತಕ್ಕದ್ದು.

(ಆ) ಹಂಚಿಕೆದಾರರು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತಕ್ಕೆ ಠೇವಣಿ ಇಡುವ ಹಣವನ್ನು, ವಿವರವಾದ ಯೋಜನಾ ವರದಿಯನ್ನು (ಡಿಪಿಆರ್) ಆವಿಷ್ಕರಿಸುವುದಕ್ಕೋಸ್ಕರ ಹೊಂದಾಣಿಕೆ ಮಾಡಿಕೊಳ್ಳಲಾಗುವುದು.

3 ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತವು ಯೋಜನಾ ವರದಿಗೆ ತಾಂತ್ರಿಕ ಅನುಮೋದನೆ ಕೊಟ್ಟ ಆರು ತಿಂಗಳ ಒಳಗಾಗಿ ಫೈನಾನ್ಸಿಯಲ್ ಕ್ಲೋಷರ್‌ನ್ನು ಸಾಧಿಸತಕ್ಕದ್ದು.

4 ಫೈನಾನ್ಸಿಯಲ್ ಕ್ಲೋಷರ್‌ನ್ನು ಸಾಧಿಸಿದ 24 ತಿಂಗಳ ಒಳಗಾಗಿ ಯೋಜನೆಯನ್ನು ಮುಗಿಸುವ ನಿಟ್ಟಿನಲ್ಲಿ ಹಂಚಿಕೆದಾರರು ಕಾರ್ಯಪ್ರವೃತ್ತರಾಗತಕ್ಕದ್ದು.

5 ಮೇಲೆ ತಿಳಿಸಿದ 2, 3 ಮತ್ತು 4 ಅಂಶಗಳ ಯೋಜನಾ ಅನುಷ್ಠಾನ ಮಾಡಲು ಸಫಲವಾಗದಿದ್ದಲ್ಲಿ ಈ ಹಂಚಿಕೆಯು ತಂತಾನೇ ಯಾವ ಮುನ್ಸೂಚನೆಯನ್ನೂ ನೀಡದೆ ರದ್ದಾಗುವುದೆಂದು ತಿಳಿಯತಕ್ಕದ್ದು.

6 ಯೋಜನಾ ಅಭಿವೃದ್ಧಿದಾರರು ವಿದ್ಯುತ್ತನ್ನು ಮೂರನೆಯವರಿಗೆ ಮಾರಾಟ ಮಾಡುವ ಸಂದರ್ಭದಲ್ಲಿ ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತದೊಂದಿಗೆ ವೀಲಿಂಗ್ ಅಂಡ್ ಬ್ಯಾಂಕಿಂಗ್ ಒಡಂಬಡಿಕೆ ಮಾಡಿಕೊಳ್ಳಲು ಮತ್ತು ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತಕ್ಕೆ ವಿದ್ಯುತ್ತನ್ನು ಮಾರಾಟ ಮಾಡುವ ಸಂದರ್ಭದಲ್ಲಿ ವಿದ್ಯುತ್ ಖರೀದಿ ಒಡಂಬಡಿಕೆ (ಪಿಪಿಎ) ಮಾಡಿಕೊಳ್ಳಲು ಅನುಮತಿ ನೀಡಲಾಗಿದೆ.

7 ಈ ವಿಷಯದಲ್ಲಿ ಹಂಚಿಕೆದಾರರು ರಾಜ್ಯ ಮತ್ತು ಜಿಲ್ಲಾ ಮಟ್ಟಕ್ಕೆ ಸಂಬಂಧಿಸಿದ ಅಧಿಕಾರಿಗಳ ಸಹಾಯ / ಸಹಕಾರವನ್ನು ಪಡೆದು ನಿಗದಿತ ಅವಧಿಯೊಳಗೆ ಯೋಜನಾ ಅನುಷ್ಠಾನ ಪೂರ್ಣಗೊಳಿಸತಕ್ಕದ್ದು.

8. ಈ ಕಿರು ಜಲ ವಿದ್ಯುತ್ ಯೋಜನೆಯ ಸ್ಥಳದಲ್ಲಿ ಯಾವುದಾದರು ಸರ್ಕಾರಿ ಜಲ ವಿದ್ಯುತ್ / ನೀರಾವರಿ / ಕುಡಿಯುವ ನೀರಿನ ಯೋಜನೆಗಳು ಬಂದಲ್ಲಿ ಸರ್ಕಾರಿ ಯೋಜನೆಗಳಿಗೆ ಮೊದಲ ಆದ್ಯತೆ ದೊರಕುವುದು ಹಾಗೂ ಈ ಯೋಜನೆಗೆ ಯಾವುದಾದರೂ ಇತರೆ ಯೋಜನೆಗಳಿಂದ ಧಕ್ಕೆಯಾದ್ದಲ್ಲಿ ಯಾವುದೇ ಪರಿಹಾರವನ್ನು ಅಭಿವೃದ್ಧಿದಾರರು ನಿರೀಕ್ಷಿಸುವಂತಿಲ್ಲ.

9. ಸ್ಥಳೀಯವಾಗಿ ಉದ್ಭವಿಸುವ ಯಾವುದಾದರೂ ಆಕ್ಷೇಪಣೆಗಳಿಗೆ ಅಭಿವೃದ್ಧಿದಾರರೇ ಸಂಪೂರ್ಣವಾಗಿ ಹೊಣೆಗಾರರಾಗಿರುತ್ತಾರೆ.

10 ಕರ್ನಾಟಕ ವಿದ್ಯುತ್ ನಿಗಮ ನಿಯಮಿತದ ಯಾವುದೇ ಯೋಜನೆಗಳಿಂದಾಗಿ ಸದರಿ ಯೋಜನೆಯು ಮುಳುಗಡೆಯಾದಲ್ಲಿ, ಒದಗಬಹುದಾದ ಸಂಪೂರ್ಣ ತೊಂದರೆಗಳಿಗೆ ಅಭಿವೃದ್ಧಿದಾರರೇ ಪೂರ್ಣ ಜವಾಬ್ದಾರರಾಗಿರುತ್ತಾರೆ.

11 ಸದರಿ ಆದೇಶವನ್ನು ರದ್ದು ಪಡಿಸುವುದು/ಮಾರ್ಪಾಡು ಮಾಡುವ ಅಧಿಕಾರವನ್ನು ಸರ್ಕಾರವು ಹೊಂದಿರುತ್ತದೆ.

12 ಡಿ.ಪಿ.ಆರ್. ತಯಾರು ಮಾಡಿದ ಮೇಲೆ ಕ್ರೆಡಲ್ ಸಂಸ್ಥೆಯು ಪರಿಶೀಲಿಸಿದ ನಂತರ ಇತರ ಸಂಬಂಧಿಸಿದ ಇಲಾಖೆಗಳಿಗೆ ಡಿ.ಪಿ.ಆರ್. ಸಲ್ಲಿಸುವುದು ಹಾಗೂ ತದನಂತರ ತಾಂತ್ರಿಕ ಅನುಮೋದನೆಗಾಗಿ ಕ್ರೆಡಲ್‌ಗೆ ಅರ್ಜಿ ಸಲ್ಲಿಸತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1323 **ಎಸ್.ಜೆ. ಸಂಪತ್ ಕುಮಾರ್**

ಸರ್ಕಾರದ ಅಧೀನ ಕಾರ್ಯದರ್ಶಿ, ಇಂಧನ ಇಲಾಖೆ.

**ವಿಷಯ:** ಮೆ:: Chamundeshwari Energy Pvt. Ltd. ಕಂಪನಿಗೆ 3.00 ಮೆಗಾ ವ್ಯಾಟ್ ಸಾಮರ್ಥ್ಯದ ಚಿಕೋತನಹಾಡಿ ಕಿರು ಜಲ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡುವ ಬಗ್ಗೆ.

**ಓದಲಾಗಿದೆ:** 1 ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತ ಸಂಸ್ಥೆಯ ವ್ಯವಸ್ಥಾಪಕ ನಿರ್ದೇಶಕರ ಪತ್ರ ಸಂಖ್ಯೆ: ಕೆಆರ್‌ಇಡಿ/06/ಚಿಕೋತನಹಾಡಿ/07/2965 ದಿನಾಂಕ: 24/25.01.2008.

2 ದಿನಾಂಕ: 13.2.2009 ರಂದು ನಡೆದ ಹಂಚಿಕೆ ಸಮಿತಿ ಸಭೆಯ ನಡವಳಿಗಳು.

**ಪ್ರಸ್ತಾವನೆ :–**

ಮೇಲೆ ಓದಲಾದ ಕ್ರಮ ಸಂಖ್ಯೆ (1) ರ ಪತ್ರದಲ್ಲಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ವ್ಯವಸ್ಥಾಪಕ ನಿರ್ದೇಶಕರು ಮೆ:: Chamundeshwari Energy Pvt. Ltd. ಕಂಪನಿಗೆ ಉಡುಪಿ ಜಿಲ್ಲೆಯ ಕುಂದಾಪುರ

ತಾಲ್ಲೂಕಿನ ಚಿಕೋತನಹಾಡಿ ಗ್ರಾಮದ ಬಳಿ ಕುಬ್ಜಾ ನದಿಗೆ ಅಡ್ಡಲಾಗಿ 3.00 ಮೆಗಾ ವ್ಯಾಟ್ ಸಾಮರ್ಥ್ಯದ ಚಿಕೋತನಹಾಡಿ ಕಿರು ಜಲ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡುವಂತೆ ಸರ್ಕಾರಕ್ಕೆ ಶಿಫಾರಸ್ಸು ಮಾಡಿರುತ್ತಾರೆ.

ಮೇಲೆ ಓದಲಾದ ಕ್ರಮ ಸಂಖ್ಯೆ (2) ರ ಹಂಚಿಕೆ ಸಮಿತಿ ಸಭೆಯಲ್ಲಿ ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಅನುಮೋದನೆ ನೀಡಲಾಗಿದೆ. ಆದುದರಿಂದ, ಈ ಕೆಳಗಿನಂತೆ ಆದೇಶಿಸಲಾಗಿದೆ :–

**ಸರ್ಕಾರದ ಆದೇಶ ಸಂಖ್ಯೆ: ಇಎನ್ 44 ಎನ್‌ಸಿಇ 2008, ಬೆಂಗಳೂರು, ದಿನಾಂಕ: 19ನೇ ಮೇ 2009.**

ಮೆ:: Chamundeshwari Energy Pvt. Ltd. ಕಂಪನಿಗೆ ಉಡುಪಿ ಜಿಲ್ಲೆಯ ಕುಂದಾಪುರ ತಾಲ್ಲೂಕಿನ ಚಿಕೋತನಹಾಡಿ ಗ್ರಾಮದ ಬಳಿ ಕುಬ್ಜಾ ನದಿಗೆ ಅಡ್ಡಲಾಗಿ 3.00 ಮೆಗಾ ವ್ಯಾಟ್ ಸಾಮರ್ಥ್ಯದ ಚಿಕೋತನಹಾಡಿ ಕಿರು ಜಲ ವಿದ್ಯುತ್ ಯೋಜನೆಯನ್ನು (**Latitude**: 13 40'08", **Longitude**: 76 52'40") ಈ ಕೆಳಗಿನ ನಿಬಂಧನೆಗೊಳಪಟ್ಟು ಹಂಚಿಕೆ ಮಾಡಲಾಗಿದೆ:–

1(ಅ) ಸದರಿ ಯೋಜನೆಯಿಂದ ಕೆಳ ತೊರೆ ಮತ್ತು ಮೇಲ್ತೊರೆ ಯೋಜನೆಗಳಿಗೆ ಯಾವುದೇ ಹಾನಿಯಾಗಬಾರದು.

(ಆ) ಹಂಚಿಕೆದಾರರು ಈ ಆದೇಶ ಹೊರಡಿಸಿದ ಮೂರು ತಿಂಗಳ ಒಳಗಾಗಿ ಸರ್ಕಾರದೊಂದಿಗೆ ಒಡಂಬಡಿಕೆಯನ್ನು ಮಾಡಿಕೊಳ್ಳತಕ್ಕದ್ದು. ಇಲ್ಲದಿದ್ದಲ್ಲಿ, ಈ ಹಂಚಿಕೆ ತಂತಾನೇ ರದ್ದಾಗುವುದು. ನಂತರ, ಕಂಪನಿಯು ಹಂಚಿಕೆಗೋಸ್ಕರ ಪುನಃ ಹೊಸದಾಗಿ ಅರ್ಜಿ ಸಲ್ಲಿಸತಕ್ಕದ್ದು. ಯಾವ ಕಾರಣಕ್ಕೂ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತವು ಸ್ವೀಕರಿಸಿದ ಅರ್ಜಿ ಪರಿಷ್ಕರಣಾ ಶುಲ್ಕವನ್ನು ಹಿಂದಿರುಗಿಸಲಾಗುವುದಿಲ್ಲ.

(ಇ) ಒಡಂಬಡಿಕೆಯನ್ನು ರೂ. 400.00ರ ಛಾಪಾ ಕಾಗದದ ಮೇಲೆ ಮಾಡಿಕೊಂಡು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದವರಿಗೆ ಕಳುಹಿಸಿ ಪ್ರಮಾಣೀಕರಿಸಿ ಸರ್ಕಾರಕ್ಕೆ ಕಳುಹಿಸಿಕೊಡತಕ್ಕದ್ದು.

(ಈ) ಈ ಒಡಂಬಡಿಕೆಯನ್ನು ಮಾಡಿಕೊಳ್ಳುವ ಮೊದಲು ಯೋಜನಾ ಅಭಿವೃದ್ಧಿದಾರರು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮತಕ್ಕೆ ವಿವರವಾದ ಯೋಜನಾ ವರದಿಯನ್ನು (ಡಿ.ಪಿ.ಆರ್) ಪರಿಷ್ಕರಿಸಲು ಮೆಗಾವಾಟ್ ಒಂದಕ್ಕೆ ರೂ. 25,000.00 ದಂತೆ ರೂ. 1.00 ಲಕ್ಷಕ್ಕೆ ಕಡಿಮೆ ಇಲ್ಲದಂತೆ ಪಾವತಿಸತಕ್ಕದ್ದು.

2(ಅ) ಯೋಜನಾ ಅಭಿವೃದ್ಧಿದಾರರು ಸಂಬಂಧಪಟ್ಟ ಎಲ್ಲಾ ಇಲಾಖೆಗಳಿಂದಲೂ ಅಂದರೆ ಜಲಸಂಪನ್ಮೂಲ ಇಲಾಖೆ, ಅರಣ್ಯ, ಜೀವಿಶಾಸ್ತ್ರ & ಪರಿಸರ ಇಲಾಖೆ, ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತ, ಕರ್ನಾಟಕ ವಿದ್ಯುತ್ ನಿಗಮ ನಿಯಮಿತ, ಕರ್ನಾಟಕ ಮಾಲಿನ್ಯ ನಿಯಂತ್ರಣ ಮಂಡಳಿ ಮತ್ತು ಕಂದಾಯ ಇಲಾಖೆಗಳಿಂದ ಕ್ಲಿಯರೆನ್ಸ್‌ಗಾಗಿ ಅರ್ಜಿ ಸಲ್ಲಿಸತಕ್ಕದ್ದು. ಒಡಂಬಡಿಕೆ ಮಾಡಿಕೊಂಡ ಒಂದು ವರ್ಷದೊಳಗಾಗಿ ವಿವರವಾದ ಯೋಜನಾ ವರದಿಯನ್ನು ಸಲ್ಲಿಸತಕ್ಕದ್ದು.

(ಆ) ಹಂಚಿಕೆದಾರರು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತಕ್ಕೆ ಠೇವಣಿ ಇಡುವ ಹಣವನ್ನು, ವಿವರವಾದ ಯೋಜನಾ ವರದಿಯನ್ನು (ಡಿಪಿಆರ್) ಆವಿಷ್ಕರಿಸುವುದಕ್ಕೋಸ್ಕರ ಹೊಂದಾಣಿಕೆ ಮಾಡಿಕೊಳ್ಳಲಾಗುವುದು.

3 ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತವು ಯೋಜನಾ ವರದಿಗೆ ತಾಂತ್ರಿಕ ಅನುಮೋದನೆ ಕೊಟ್ಟ ಆರು ತಿಂಗಳ ಒಳಗಾಗಿ ಫೈನಾನ್ಸಿಯಲ್ ಕ್ಲೋಷರ್‌ನ್ನು ಸಾಧಿಸತಕ್ಕದ್ದು.

4 ಫೈನಾನ್ಸಿಯಲ್ ಕ್ಲೋಷರ್‌ನ್ನು ಸಾಧಿಸಿದ 24 ತಿಂಗಳ ಒಳಗಾಗಿ ಯೋಜನೆಯನ್ನು ಮುಗಿಸುವ ನಿಟ್ಟಿನಲ್ಲಿ ಹಂಚಿಕೆದಾರರು ಕಾರ್ಯಪ್ರವೃತ್ತರಾಗತಕ್ಕದ್ದು.

5 ಮೇಲೆ ತಿಳಿಸಿದ 2, 3 ಮತ್ತು 4 ಅಂಶಗಳ ಯೋಜನಾ ಅನುಷ್ಠಾನ ಮಾಡಲು ಸಫಲವಾಗದಿದ್ದಲ್ಲಿ ಈ ಹಂಚಿಕೆಯು ತಂತಾನೇ ಯಾವ ಮುನ್ಸೂಚನೆಯನ್ನೂ ನೀಡದೆ ರದ್ದಾಗುವುದೆಂದು ತಿಳಿಯತಕ್ಕದ್ದು.

6 ಯೋಜನಾ ಅಭಿವೃದ್ಧಿದಾರರು ವಿದ್ಯುತ್ತನ್ನು ಮೂರನೆಯವರಿಗೆ ಮಾರಾಟ ಮಾಡುವ ಸಂದರ್ಭದಲ್ಲಿ ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತದೊಂದಿಗೆ ವೀಲಿಂಗ್ ಅಂಡ್ ಬ್ಯಾಂಕಿಂಗ್ ಒಡಂಬಡಿಕೆ ಮಾಡಿಕೊಳ್ಳಲು ಮತ್ತು ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತಕ್ಕೆ ವಿದ್ಯುತ್ತನ್ನು ಮಾರಾಟ ಮಾಡುವ ಸಂದರ್ಭದಲ್ಲಿ ವಿದ್ಯುತ್ ಖರೀದಿ ಒಡಂಬಡಿಕೆ (ಪಿಪಿಎ) ಮಾಡಿಕೊಳ್ಳಲು ಅನುಮತಿ ನೀಡಲಾಗಿದೆ.

7 ಈ ವಿಷಯದಲ್ಲಿ ಹಂಚಿಕೆದಾರರು ರಾಜ್ಯ ಮತ್ತು ಜಿಲ್ಲಾ ಮಟ್ಟಕ್ಕೆ ಸಂಬಂಧಿಸಿದ ಅಧಿಕಾರಿಗಳ ಸಹಾಯ / ಸಹಕಾರವನ್ನು ಪಡೆದು ನಿಗದಿತ ಅವಧಿಯೊಳಗೆ ಯೋಜನಾ ಅನುಷ್ಠಾನ ಪೂರ್ಣಗೊಳಿಸತಕ್ಕದ್ದು.

8. ಈ ಕಿರು ಜಲ ವಿದ್ಯುತ್ ಯೋಜನೆಯ ಸ್ಥಳದಲ್ಲಿ ಯಾವುದಾದರು ಸರ್ಕಾರಿ ಜಲ ವಿದ್ಯುತ್ / ನೀರಾವರಿ / ಕುಡಿಯುವ ನೀರಿನ ಯೋಜನೆಗಳು ಬಂದಲ್ಲಿ ಸರ್ಕಾರಿ ಯೋಜನೆಗಳಿಗೆ ಮೊದಲ ಆದ್ಯತೆ ದೊರಕುವುದು ಹಾಗೂ ಈ ಯೋಜನೆಗೆ ಯಾವುದಾದರೂ ಇತರೆ ಯೋಜನೆಗಳಿಂದ ಧಕ್ಕೆಯಾದ್ದಲ್ಲಿ ಯಾವುದೇ ಪರಿಹಾರವನ್ನು ಅಭಿವೃದ್ಧಿದಾರರು ನಿರೀಕ್ಷಿಸುವಂತಿಲ್ಲ.

9. ಸ್ಥಳೀಯವಾಗಿ ಉದ್ಭವಿಸುವ ಯಾವುದಾದರೂ ಆಕ್ಷೇಪಣೆಗಳಿಗೆ ಅಭಿವೃದ್ಧಿದಾರರೇ ಸಂಪೂರ್ಣವಾಗಿ ಹೊಣೆಗಾರರಾಗಿರುತ್ತಾರೆ.

10 ಕರ್ನಾಟಕ ವಿದ್ಯುತ್ ನಿಗಮ ನಿಯಮಿತದ ಯಾವುದೇ ಯೋಜನೆಗಳಿಂದಾಗಿ ಸದರಿ ಯೋಜನೆಯು ಮುಳುಗಡೆಯಾದಲ್ಲಿ, ಒದಗಬಹುದಾದ ಸಂಪೂರ್ಣ ತೊಂದರೆಗಳಿಗೆ ಅಭಿವೃದ್ಧಿದಾರರೇ ಪೂರ್ಣ ಜವಾಬ್ದಾರರಾಗಿರುತ್ತಾರೆ.

11 ಸದರಿ ಆದೇಶವನ್ನು ರದ್ದು ಪಡಿಸುವುದು/ಮಾರ್ಪಾಡು ಮಾಡುವ ಅಧಿಕಾರವನ್ನು ಸರ್ಕಾರವು ಹೊಂದಿರುತ್ತದೆ.

12 ಡಿ.ಪಿ.ಆರ್. ತಯಾರು ಮಾಡಿದ ಮೇಲೆ ಕ್ರೆಡಲ್ ಸಂಸ್ಥೆಯು ಪರಿಶೀಲಿಸಿದ ನಂತರ ಇತರ ಸಂಬಂಧಿಸಿದ ಇಲಾಖೆಗಳಿಗೆ ಡಿ.ಪಿ.ಆರ್. ಸಲ್ಲಿಸುವುದು ಹಾಗೂ ತದನಂತರ ತಾಂತ್ರಿಕ ಅನುಮೋದನೆಗಾಗಿ ಕ್ರೆಡಲ್‌ಗೆ ಅರ್ಜಿ ಸಲ್ಲಿಸತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1324

**ಎಸ್.ಜಿ. ಸಂಪತ್ ಕುಮಾರ್**

ಸರ್ಕಾರದ ಅಧೀನ ಕಾರ್ಯದರ್ಶಿ, ಇಂಧನ ಇಲಾಖೆ.

**ವಿಷಯ:** ಮೆ:: Disha Power Corporation Pvt Ltd. ಕಂಪನಿಗೆ 6.00 ಮೆಗಾ ವ್ಯಾಟ್ ಸಾಮರ್ಥ್ಯದ ಶ್ರೀ ಅಮೃತಾನಾರಾಯಣ ಸ್ವಾಮಿ ಕಿರು ಜಲ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡುವ ಬಗ್ಗೆ.

**ಓದಲಾಗಿದೆ:** 1 ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತ ಸಂಸ್ಥೆಯ ವ್ಯವಸ್ಥಾಪಕ ನಿರ್ದೇಶಕರ ಪತ್ರ ಸಂಖ್ಯೆ: ಕೆಆರ್ಇಡಿ/06/ಶ್ರೀ ಅಮೃತಾನಾರಾಯಣ ಸ್ವಾಮಿ/07/2970 ದಿನಾಂಕ: 24/25.01.2008.

2 ದಿನಾಂಕ: 13.2.2009 ರಂದು ನಡೆದ ಹಂಚಿಕೆ ಸಮಿತಿ ಸಭೆಯ ನಡವಳಿಗಳು.

**ಪ್ರಸ್ತಾವನೆ :–**

ಮೇಲೆ ಓದಲಾದ ಕ್ರಮ ಸಂಖ್ಯೆ (1) ರ ಪತ್ರದಲ್ಲಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ವ್ಯವಸ್ಥಾಪಕ ನಿರ್ದೇಶಕರು ಮೆ:: Disha Power Corporation Pvt Ltd. ಕಂಪನಿಗೆ ರಾಮನಗರ ಜಿಲ್ಲೆಯ ರಾಮನಗರ ತಾಲ್ಲೂಕಿನ ತಿಪ್ಪೂರು ಗ್ರಾಮದ ವೃಷಬಾವತಿ ನದಿಗೆ ಅಡ್ಡಲಾಗಿ 6.00 ಮೆಗಾ ವ್ಯಾಟ್ ಸಾಮರ್ಥ್ಯದ ಶ್ರೀ ಅಮೃತಾನಾರಾಯಣ ಸ್ವಾಮಿ ಕಿರು ಜಲ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡುವಂತೆ ಸರ್ಕಾರಕ್ಕೆ ಶಿಫಾರಸ್ಸು ಮಾಡಿರುತ್ತಾರೆ.

ಮೇಲೆ ಓದಲಾದ ಕ್ರಮ ಸಂಖ್ಯೆ (2) ರ ಹಂಚಿಕೆ ಸಮಿತಿ ಸಭೆಯಲ್ಲಿ ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಅನುಮೋದನೆ ನೀಡಲಾಗಿದೆ. ಆದುದರಿಂದ, ಈ ಕೆಳಗಿನಂತೆ ಆದೇಶಿಸಲಾಗಿದೆ :–

**ಸರ್ಕಾರದ ಆದೇಶ ಸಂಖ್ಯೆ: ಇಎನ್ 48 ಎನ್‌ಸಿಇ 2008, ಬೆಂಗಳೂರು, ದಿನಾಂಕ: 19ನೇ ಮೇ 2009.**

ಮೆ:: Disha Power Corporation Pvt Ltd. ಕಂಪನಿಗೆ ರಾಮನಗರ ಜಿಲ್ಲೆಯ ರಾಮನಗರ ತಾಲ್ಲೂಕಿನ ತಿಪ್ಪೂರು ಗ್ರಾಮದ ವೃಷಬಾವತಿ ನದಿಗೆ ಅಡ್ಡಲಾಗಿ 6.00 ಮೆಗಾ ವ್ಯಾಟ್ ಸಾಮರ್ಥ್ಯದ ಶ್ರೀ ಅಮೃತಾನಾರಾಯಣ ಸ್ವಾಮಿ ಕಿರು ಜಲ ವಿದ್ಯುತ್ ಯೋಜನೆಯನ್ನು ಈ ಕೆಳಗಿನ ನಿಬಂಧನೆಗೊಳಪಟ್ಟು ಹಂಚಿಕೆ ಮಾಡಲಾಗಿದೆ:–

1(ಅ) ಸದರಿ ಯೋಜನೆಯಿಂದ ಕೆಳ ತೊರೆ ಮತ್ತು ಮೇಲ್ತೊರೆ ಯೋಜನೆಗಳಿಗೆ ಯಾವುದೇ ಹಾನಿಯಾಗಬಾರದು.

(ಆ) ಹಂಚಿಕೆದಾರರು ಈ ಆದೇಶ ಹೊರಡಿಸಿದ ಮೂರು ತಿಂಗಳ ಒಳಗಾಗಿ ಸರ್ಕಾರದೊಂದಿಗೆ ಒಡಂಬಡಿಕೆಯನ್ನು ಮಾಡಿಕೊಳ್ಳತಕ್ಕದ್ದು. ಇಲ್ಲದಿದ್ದಲ್ಲಿ, ಈ ಹಂಚಿಕೆ ತಂತಾನೇ ರದ್ದಾಗುವುದು. ನಂತರ, ಕಂಪನಿಯು ಹಂಚಿಕೆಗೋಸ್ಕರ ಪುನಃ ಹೊಸದಾಗಿ ಅರ್ಜಿ ಸಲ್ಲಿಸತಕ್ಕದ್ದು. ಯಾವ ಕಾರಣಕ್ಕೂ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತವು ಸ್ವೀಕರಿಸಿದ ಅರ್ಜಿ ಪರಿಷ್ಕರಣಾ ಶುಲ್ಕವನ್ನು ಹಿಂದಿರುಗಿಸಲಾಗುವುದಿಲ್ಲ.

(ಇ) ಒಡಂಬಡಿಕೆಯನ್ನು ರೂ. 400.00ರ ಛಾಪಾ ಕಾಗದದ ಮೇಲೆ ಮಾಡಿಕೊಂಡು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದವರಿಗೆ ಕಳುಹಿಸಿ ಪ್ರಮಾಣೀಕರಿಸಿ ಸರ್ಕಾರಕ್ಕೆ ಕಳುಹಿಸಿಕೊಡತಕ್ಕದ್ದು.

(ಈ) ಸರ್ಕಾರದೊಂದಿಗೆ ಒಡಂಬಡಿಕೆಯನ್ನು ಮಾಡಿಕೊಳ್ಳುವ ಮೊದಲು ಎಲ್ಲಾ ದಾಖಲಾತಿಗಳನ್ನು ಕ್ರೆಡಲ್‌ಗೆ ಸಲ್ಲಿಸತಕ್ಕದ್ದು.

(ಉ) ಈ ಒಡಂಬಡಿಕೆಯನ್ನು ಮಾಡಿಕೊಳ್ಳುವ ಮೊದಲು ಯೋಜನಾ ಅಭಿವೃದ್ಧಿದಾರರು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮತಕ್ಕೆ ವಿವರವಾದ ಯೋಜನಾ ವರದಿಯನ್ನು (ಡಿ.ಪಿ.ಆರ್) ಪರಿಷ್ಕರಿಸಲು ಮೆಗಾವಾಟ್ ಒಂದಕ್ಕೆ ರೂ. 25,000.00 ದಂತೆ ರೂ. 1.00 ಲಕ್ಷಕ್ಕೆ ಕಡಿಮೆ ಇಲ್ಲದಂತೆ ಪಾವತಿಸತಕ್ಕದ್ದು.

2(ಅ) ಯೋಜನಾ ಅಭಿವೃದ್ಧಿದಾರರು ಸಂಬಂಧಪಟ್ಟ ಎಲ್ಲಾ ಇಲಾಖೆಗಳಿಂದಲೂ ಅಂದರೆ ಜಲಸಂಪನ್ಮೂಲ ಇಲಾಖೆ, ಅರಣ್ಯ, ಜೀವಿಶಾಸ್ತ್ರ & ಪರಿಸರ ಇಲಾಖೆ, ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತ, ಕರ್ನಾಟಕ ವಿದ್ಯುತ್ ನಿಗಮ ನಿಯಮಿತ, ಕರ್ನಾಟಕ ಮಾಲಿನ್ಯ ನಿಯಂತ್ರಣ ಮಂಡಳಿ ಮತ್ತು ಕಂದಾಯ ಇಲಾಖೆಗಳಿಂದ ಕ್ಲಿಯರೆನ್ಸ್‌ಗಾಗಿ ಅರ್ಜಿ ಸಲ್ಲಿಸತಕ್ಕದ್ದು. ಒಡಂಬಡಿಕೆ ಮಾಡಿಕೊಂಡ ಒಂದು ವರ್ಷದೊಳಗಾಗಿ ವಿವರವಾದ ಯೋಜನಾ ವರದಿಯನ್ನು ಸಲ್ಲಿಸತಕ್ಕದ್ದು.

(ಆ) ಹಂಚಿಕೆದಾರರು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತಕ್ಕೆ ಠೇವಣಿ ಇಡುವ ಹಣವನ್ನು, ವಿವರವಾದ ಯೋಜನಾ ವರದಿಯನ್ನು (ಡಿಪಿಆರ್) ಆವಿಷ್ಕರಿಸುವುದಕ್ಕೋಸ್ಕರ ಹೊಂದಾಣಿಕೆ ಮಾಡಿಕೊಳ್ಳಲಾಗುವುದು.

3 ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತವು ಯೋಜನಾ ವರದಿಗೆ ತಾಂತ್ರಿಕ ಅನುಮೋದನೆ ಕೊಟ್ಟ ಆರು ತಿಂಗಳ ಒಳಗಾಗಿ ಫೈನಾನ್ಸಿಯಲ್ ಕ್ಲೋಷರ್‌ನ್ನು ಸಾಧಿಸತಕ್ಕದ್ದು.

4 ಫೈನಾನ್ಸಿಯಲ್ ಕ್ಲೋಷರ್‌ನ್ನು ಸಾಧಿಸಿದ 24 ತಿಂಗಳ ಒಳಗಾಗಿ ಯೋಜನೆಯನ್ನು ಮುಗಿಸುವ ನಿಟ್ಟಿನಲ್ಲಿ ಹಂಚಿಕೆದಾರರು ಕಾರ್ಯಪ್ರವೃತ್ತರಾಗತಕ್ಕದ್ದು.

5 ಮೇಲೆ ತಿಳಿಸಿದ 2, 3 ಮತ್ತು 4 ಅಂಶಗಳ ಯೋಜನಾ ಅನುಷ್ಠಾನ ಮಾಡಲು ಸಫಲವಾಗದಿದ್ದಲ್ಲಿ ಈ ಹಂಚಿಕೆಯು ತಂತಾನೇ ಯಾವ ಮುನ್ಸೂಚನೆಯನ್ನೂ ನೀಡದೆ ರದ್ದಾಗುವುದೆಂದು ತಿಳಿಯತಕ್ಕದ್ದು.

6 ಯೋಜನಾ ಅಭಿವೃದ್ಧಿದಾರರು ವಿದ್ಯುತ್ತನ್ನು ಮೂರನೆಯವರಿಗೆ ಮಾರಾಟ ಮಾಡುವ ಸಂದರ್ಭದಲ್ಲಿ ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತದೊಂದಿಗೆ ವೀಲಿಂಗ್ ಅಂಡ್ ಬ್ಯಾಂಕಿಂಗ್ ಒಡಂಬಡಿಕೆ ಮಾಡಿಕೊಳ್ಳಲು ಮತ್ತು ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತಕ್ಕೆ ವಿದ್ಯುತ್ತನ್ನು ಮಾರಾಟ ಮಾಡುವ ಸಂದರ್ಭದಲ್ಲಿ ವಿದ್ಯುತ್ ಖರೀದಿ ಒಡಂಬಡಿಕೆ (ಪಿಪಿಎ) ಮಾಡಿಕೊಳ್ಳಲು ಅನುಮತಿ ನೀಡಲಾಗಿದೆ.

7 ಈ ವಿಷಯದಲ್ಲಿ ಹಂಚಿಕೆದಾರರು ರಾಜ್ಯ ಮತ್ತು ಜಿಲ್ಲಾ ಮಟ್ಟಕ್ಕೆ ಸಂಬಂಧಿಸಿದ ಅಧಿಕಾರಿಗಳ ಸಹಾಯ / ಸಹಕಾರವನ್ನು ಪಡೆದು ನಿಗದಿತ ಅವಧಿಯೊಳಗೆ ಯೋಜನಾ ಅನುಷ್ಠಾನ ಪೂರ್ಣಗೊಳಿಸತಕ್ಕದ್ದು.

8. ಈ ಕಿರು ಜಲ ವಿದ್ಯುತ್ ಯೋಜನೆಯ ಸ್ಥಳದಲ್ಲಿ ಯಾವುದಾದರು ಸರ್ಕಾರಿ ಜಲ ವಿದ್ಯುತ್ / ನೀರಾವರಿ / ಕುಡಿಯುವ ನೀರಿನ ಯೋಜನೆಗಳು ಬಂದಲ್ಲಿ ಸರ್ಕಾರಿ ಯೋಜನೆಗಳಿಗೆ ಮೊದಲ ಆದ್ಯತೆ ದೊರಕುವುದು ಹಾಗೂ ಈ ಯೋಜನೆಗೆ ಯಾವುದಾದರೂ ಇತರೆ ಯೋಜನೆಗಳಿಂದ ಧಕ್ಕೆಯಾದ್ದಲ್ಲಿ ಯಾವುದೇ ಪರಿಹಾರವನ್ನು ಅಭಿವೃದ್ಧಿದಾರರು ನಿರೀಕ್ಷಿಸುವಂತಿಲ್ಲ.

9. ಸ್ಥಳೀಯವಾಗಿ ಉದ್ಭವಿಸುವ ಯಾವುದಾದರೂ ಆಕ್ಷೇಪಣೆಗಳಿಗೆ ಅಭಿವೃದ್ಧಿದಾರರೇ ಸಂಪೂರ್ಣವಾಗಿ ಹೊಣೆಗಾರರಾಗಿರುತ್ತಾರೆ.

10 ಕರ್ನಾಟಕ ವಿದ್ಯುತ್ ನಿಗಮ ನಿಯಮಿತದ ಯಾವುದೇ ಯೋಜನೆಗಳಿಂದಾಗಿ ಸದರಿ ಯೋಜನೆಯು ಮುಳುಗಡೆಯಾದಲ್ಲಿ, ಒದಗಬಹುದಾದ ಸಂಪೂರ್ಣ ತೊಂದರೆಗಳಿಗೆ ಅಭಿವೃದ್ಧಿದಾರರೇ ಪೂರ್ಣ ಜವಾಬ್ದಾರರಾಗಿರುತ್ತಾರೆ.

11 ಸದರಿ ಆದೇಶವನ್ನು ರದ್ದು ಪಡಿಸುವುದು/ಮಾರ್ಪಾಡು ಮಾಡುವ ಅಧಿಕಾರವನ್ನು ಸರ್ಕಾರವು ಹೊಂದಿರುತ್ತದೆ.

12 ಡಿ.ಪಿ.ಆರ್. ತಯಾರು ಮಾಡಿದ ಮೇಲೆ ಕ್ರೆಡಲ್ ಸಂಸ್ಥೆಯು ಪರಿಶೀಲಿಸಿದ ನಂತರ ಇತರ ಸಂಬಂಧಿಸಿದ ಇಲಾಖೆಗಳಿಗೆ ಡಿ.ಪಿ.ಆರ್. ಸಲ್ಲಿಸುವುದು ಹಾಗೂ ತದನಂತರ ತಾಂತ್ರಿಕ ಅನುಮೋದನೆಗಾಗಿ ಕ್ರೆಡಲ್‌ಗೆ ಅರ್ಜಿ ಸಲ್ಲಿಸತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1325

**ಎಸ್.ಜೆ. ಸಂಪತ್ ಕುಮಾರ್**

ಸರ್ಕಾರದ ಅಧೀನ ಕಾರ್ಯದರ್ಶಿ, ಇಂಧನ ಇಲಾಖೆ.

**ವಿಷಯ:** ಮೆ:: Chamundeshwari Energy Pvt. Ltd. ಕಂಪನಿಗೆ 3.00 ಮೆಗಾ ವ್ಯಾಟ್ ಸಾಮರ್ಥ್ಯದ ಮುದುಗಲ್ ಕಿರು ಜಲ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡುವ ಬಗ್ಗೆ.

**ಓದಲಾಗಿದೆ:** 1 ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತ ಸಂಸ್ಥೆಯ ವ್ಯವಸ್ಥಾಪಕ ನಿರ್ದೇಶಕರ ಪತ್ರ ಸಂಖ್ಯೆ: ಕೆಆರ್‌ಇಡಿ/06/ಮುದುಗಲ್/07/2968 ದಿನಾಂಕ: 24/25.01.2008.

2 ದಿನಾಂಕ: 13.2.2009 ರಂದು ನಡೆದ ಹಂಚಿಕೆ ಸಮಿತಿ ಸಭೆಯ ನಡವಳಿಗಳು.

**ಪ್ರಸ್ತಾವನೆ :–**

ಮೇಲೆ ಓದಲಾದ ಕ್ರಮ ಸಂಖ್ಯೆ (1) ರ ಪತ್ರದಲ್ಲಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ವ್ಯವಸ್ಥಾಪಕ ನಿರ್ದೇಶಕರು ಮೆ:: Chamundeshwari Energy Pvt. Ltd. ಕಂಪನಿಗೆ ಉಡುಪಿ ಜಿಲ್ಲೆಯ ಕುಂದಾಪುರ ತಾಲ್ಲೂಕಿನ ಹಂಚೆಕಟ್ಟೆ ಗ್ರಾಮದ ಬಳಿ ಚಕ್ರಾ ನದಿಗೆ ಅಡ್ಡಲಾಗಿ 3.00 ಮೆಗಾ ವ್ಯಾಟ್ ಸಾಮರ್ಥ್ಯದ ಮುದುಗಲ್ ಕಿರು ಜಲ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡುವಂತೆ ಸರ್ಕಾರಕ್ಕೆ ಶಿಫಾರಸ್ಸು ಮಾಡಿರುತ್ತಾರೆ.

ಮೇಲೆ ಓದಲಾದ ಕ್ರಮ ಸಂಖ್ಯೆ (2) ರ ಹಂಚಿಕೆ ಸಮಿತಿ ಸಭೆಯಲ್ಲಿ ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಅನುಮೋದನೆ ನೀಡಲಾಗಿದೆ. ಆದುದರಿಂದ, ಈ ಕೆಳಗಿನಂತೆ ಆದೇಶಿಸಲಾಗಿದೆ :–

**ಸರ್ಕಾರದ ಆದೇಶ ಸಂಖ್ಯೆ: ಇಎನ್ 47 ಎನ್‌ಸಿಇ 2008, ಬೆಂಗಳೂರು, ದಿನಾಂಕ: 20.5.2009.**

ಮೆ:: Chamundeshwari Energy Pvt. Ltd. ಕಂಪನಿಗೆ ಉಡುಪಿ ಜಿಲ್ಲೆಯ ಕುಂದಾಪುರ ತಾಲ್ಲೂಕಿನ ಹಂಚೆಕಟ್ಟೆ ಗ್ರಾಮದ ಬಳಿ ಚಕ್ರಾ ನದಿಗೆ ಅಡ್ಡಲಾಗಿ 3.00 ಮೆಗಾ ವ್ಯಾಟ್ ಸಾಮರ್ಥ್ಯದ ಮುದುಗಲ್ ಕಿರು ಜಲ ವಿದ್ಯುತ್ ಯೋಜನೆಯನ್ನು (**Latitude**: 13 43'45", **Longitude**: 75 52'26")

ಈ ಕೆಳಗಿನ ನಿಬಂಧನೆಗೊಳಪಟ್ಟು ಹಂಚಿಕೆ ಮಾಡಲಾಗಿದೆ:–

1(ಅ) ಸದರಿ ಯೋಜನೆಯಿಂದ ಕೆಳ ತೊರೆ ಮತ್ತು ಮೇಲ್ತೊರೆ ಯೋಜನೆಗಳಿಗೆ ಯಾವುದೇ ಹಾನಿಯಾಗಬಾರದು.

